CPMG / KA / BG-GPO/13/2003-2005

ಸುವರ್ಣ ಕರ್ನಾಟಕ - 2006



# ಕರ್ನಾಟಕ ರಾಜ್ಯಪತ್ರ

ಅಧಿಕೃತವಾಗಿ ಪ್ರಕಟಿಸಲಾದುದು

| ಸಂಪುಟ ೧೪೦ | ಬೆಂಗಳೂರು, ಗುರುವಾರ, ಸೆಪ್ಟೆಂಬರ್ ೨೨, ೨೦೦೫ (ಭಾದ್ರಪದ ೩೧, ಶಕ ವರ್ಷ ೧೯೨೭) | ಸಂಚಿಕೆ ೩೮ |
|---|---|---|

## ಭಾಗ - ೧

## ರಾಜ್ಯ ಸರ್ಕಾರದ ಮುಖ್ಯ ಆದೇಶಗಳು ಹಾಗೂ ಸುತ್ತೋಲೆ ಮುಂತಾಗಿ ಎಲ್ಲಾ ಇಲಾಖೆಗಳಿಗೂ ಸಂಬಂಧಿಸಿದ ಆದೇಶಗಳು.

### ಇಂಧನ ಸಚಿವಾಲಯ

**ವಿಷಯ :** ಪವನ ವಿದ್ಯುತ್ ಯೋಜನೆ ಅಭಿವೃದ್ಧಿಗಾಗಿ ಹಂಚಿಕೆ ಆದೇಶ.

**ಓದಲಾಗಿದೆ :**
1. ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ: ಕೆಆರ್‌ಇಡಿ: 08: ಎಸ್‌ಡಿಪಿಎಲ್: 2005: 1373:704 ದಿನಾಂಕ: 26.7.2005 ಮತ್ತು 08.04.2005.
2. ದಿನಾಂಕ: 28.07.2005 ರಂದು ನಡೆದ ಹಂಚಿಕೆ ಸಮಿತಿ ಸಭೆಯ ನಡವಳಿಗಳು.

**ಪ್ರಸ್ತಾವನೆ:**

ಓದಲಾದ (1)ರ ಪತ್ರದಲ್ಲಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ವ್ಯವಸ್ಥಾಪಕ ನಿರ್ದೇಶಕರು ಮೆ:ಸುಜ್ಲಾನ್ ಡೆವಲಪರ್ಸ್ ಲಿಮಿಟೆಡ್, ಬೆಂಗಳೂರು ಈ ಕಂಪನಿಗೆ ಹಾಸನ ಜಿಲ್ಲೆಯಲ್ಲಿ 12.4 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಹಂಚಿಕೆ ಮಾಡುವಂತೆ ಸರ್ಕಾರಕ್ಕೆ ಶಿಫಾರಸ್ಸು ಮಾಡಿರುತ್ತಾರೆ.

ಸದರಿ ಪ್ರಸ್ತಾವನೆಯನ್ನು ಓದಲಾದ (2)ರಲ್ಲಿ ಹೇಳಿದ ಹಂಚಿಕೆ ಸಮಿತಿ ಸಭೆ ನಡವಳಿಯಲ್ಲಿನ ಪವನ ವಿದ್ಯುತ್ ಯೋಜನೆಗಳ ಹಂಚಿಕೆಗಳಲ್ಲಿನ ಕ್ರಮ ಸಂಖ್ಯೆ 3ರಲ್ಲಿ ಅನುಮೋದಿಸಿದ್ದರನ್ವಯ ಕೂಲಂಕಷವಾಗಿ ಪರಿಶೀಲಿಸಿದ್ದು ನಂತರ ಈ ಕೆಳಗಿನಂತೆ ಆದೇಶಿಸಲಾಗಿದೆ.

**ಸರ್ಕಾರಿ ಆದೇಶ ಸಂಖ್ಯೆ: ಇಎನ್ 100 ಎನ್‌ಸಿಇ 2005 ಬೆಂಗಳೂರು, ದಿನಾಂಕ: 19ನೇ ಆಗಸ್ಟ್ 2005**

ಮೆ: ಸುಜ್ಲಾನ್ ಡೆವಲಪರ್ಸ್ ಲಿಮಿಟೆಡ್, ಬೆಂಗಳೂರು ಈ ಕಂಪನಿಗೆ ಹಾಸನ ಜಿಲ್ಲೆಯಲ್ಲಿ 12.4 ಮೆ.ವ್ಯಾ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಯನ್ನು ಕೆಳಗೆ ವಿವರಿಸಿರುವಂತೆ ಈ ಕೆಳಗಿನ ನಿಬಂಧನೆಗೊಳಪಟ್ಟು ಹಂಚಿಕೆ ಮಾಡಿದೆ.

| Sl. No. | Proposed capacity in MW | Geographical area description of the project |
|---|---|---|
| 1. | 10 MW (8 nos x 1250 KW WTGs) | A North-South oriented hillock is located on the Southwest of Aladahalli village and is describe as Siegegudda State Forest. It has peak of 1151 mt Elevation. As per toposheet information the area is having boulders and the proposed area of 10 MW is bounded by the Geographical co-ordinates:<br>**Latitude:** 13$^{0}$8'15''-13$^{0}$9'25''N<br>**Longutide:** 76$^{0}$2'21''-3'11''E<br>**Peaks:**1151m elevation. |
| 2. | 2.4 MW (4 nos x 600 KW WTGs) | A Northeast-Southwest ridge located on the west of Bichenahali village has 985 mt peak elevation and the total area of 2.4 MW proposed by the company is bounded by Geographical co-odinates:<br>**Latitude:** 12$^{0}$50'19''-51$^{0}$20''N<br>**Longutide:** 76$^{0}$15'25''-16'15''E<br>**Peaks:**985m elevation. |
| Total | | |

1. ಯೋಜನಾಭಿವೃದ್ಧಿದಾರರು ಸರ್ಕಾರದೊಂದಿಗೆ ಒಡಂಬಡಿಕೆ ಮಾಡಿಕೊಳ್ಳುವ ಮೊದಲು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಮೆಗಾವ್ಯಾಟ್ ಒಂದಕ್ಕೆ ರೂ.25,000 ದಂತೆ ವಿವರವಾದ ಯೋಜನಾ ವರದಿ ಪರಿಷ್ಕರಣ ಶುಲ್ಕವನ್ನು ತುಂಬುವುದು.
2. ಈ ಆದೇಶ ಹೊರಡಿಸಿದ ದಿನಾಂಕದಿಂದ 3 ತಿಂಗಳ ಒಳಗೆ ಯೋಜನಾಭಿವೃದ್ಧಿದಾರರು ರೂ.400ರ ಛಾಪಾ ಕಾಗದದಲ್ಲಿ ಸರ್ಕಾರದೊಂದಿಗೆ ಒಡಂಬಡಿಕೆಯನ್ನು ಮಾಡಿಕೊಳ್ಳುವುದು. ತಪ್ಪಿದಲ್ಲಿ ಈ ಹಂಚಿಕೆ ಆದೇಶ ತಂತಾನೆ ರದ್ದಾಗಿದೆ ಎಂದು ಭಾವಿಸುವುದು.
3. ಹಂಚಿಕೆದಾರರು ಪೂರ್ತಿ ಒಂದು ಪವನ ವರ್ಷಕ್ಕೆ ಕಡಿಮೆ ಇಲ್ಲದಂತೆ 10 ಮೀಟರ್ ಮತ್ತು ಹಬ್‌ಹೈಟ್ ಮಟ್ಟದಲ್ಲಿ ಪವನ ವೇಗದ ಅಳತೆಯನ್ನು ಮಾಡಿಕೊಳ್ಳಬೇಕು. ಅಲ್ಲದೇ, ಕಾಲ ಕಾಲಕ್ಕೆ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದಿಂದ ಹೊರಡಿಸತಕ್ಕ ಮಾರ್ಗಸೂಚಿಗಳಿಗನುಗುಣವಾಗಿ ಮೈಕ್ರೊ ಸೈಟಿಂಗ್ ಮಾಡಿರುವ ಅಂಶಗಳನ್ನೊಳಗೊಂಡ ವಿವರವಾದ ಯೋಜನಾ ವರದಿಗಳ 3 ಪ್ರತಿಗಳನ್ನು ತಯಾರಿಸಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಮಂಡಿಸಬೇಕು. ತಾಂತ್ರಿಕ ಅವಶ್ಯಕತೆ ಮತ್ತು ಹೆಚ್ಚಿನ ವಿದ್ಯುತ್ ಉತ್ಪಾದನೆಯನ್ನು ಸೇಫ್ ನಕ್ಷೆ ಮತ್ತು ವಿಂಡ್ ಫಾರ್ಮನ ಲೇಔಟ್‌ನ ಬದಲಾವಣೆಗನುಗುಣವಾಗಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತದ ಶಿಫಾರಸ್ಸಿನಂತೆ ಇದೆ ಎಂಬುದನ್ನು ಖಾತರಿಪಡಿಸಬೇಕು.
4. ಗಾಳಿ ಚಕ್ರದ ಹಬ್ ಹೈಟಿನಲ್ಲಿ ಪವನ ವೇಗದ ಅಳತೆ ಖಾತರಿಪಡಿಸಲು ಕೆಳಗಿನ ಕೋಷ್ಟಕದಲ್ಲಿ ವಿವರಿಸಿರುವಂತೆ ಪ್ರತೀ 5 ಮೆಗಾವ್ಯಾಟ್ ಸಾಮರ್ಥ್ಯದ ಪವನ ವಿದ್ಯುತ್ ಯೋಜನೆಗೆ ಒಂದರಂತೆ ಗಾಳಿ ಕಂಬವನ್ನು (ವಿಂಡ್ ಮಾಸ್ಟ್) ಅಳವಡಿಸಬೇಕು. ಅಳತೆ ವಿವರಗಳನ್ನು ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಸಲ್ಲಿಸುವುದು.

| ಗಾಳಿ ಶಕ್ತಿ ವಿದ್ಯುತ್ತಿನ ದೂರ ಸಾಮರ್ಥ್ಯ | 5 ಮೆಗಾವ್ಯಾಟ್ ಗಾಳಿ ಯೋಜನೆಯಲ್ಲಿ ಸಾಧಾರಣ ಗಾಳಿ ಶಕ್ತಿ ವಿದ್ಯುತ್ತಿನ ಸಂಖ್ಯೆ | ಹಾಕಬೇಕಾಗಿರುವ ಗಾಳಿ ಕಂಬ (ವಿಂಡ್ ಮಾಸ್ಟ್‌ಗಳ ಸಂಖ್ಯೆ) |
|---|---|---|
| ➢ 200 ಕಿ.ವ್ಯಾ. ನಿಂದ 300 ಕಿ.ವ್ಯಾ. | 18 | 1 |
| ➢ 300 ಕಿ.ವ್ಯಾ. ನಿಂದ 500 ಕಿ.ವ್ಯಾ. | 15 | 1 |
| ➢ 500 ಕಿ.ವ್ಯಾ. ನಿಂದ 750 ಕಿ.ವ್ಯಾ. | 12 | 1 |
| ➢ 750 ಕಿ.ವ್ಯಾ. ನಿಂದ 1000 ಕಿ.ವ್ಯಾ. | 8 ರಿಂದ 10 | 1 |

5. ಯೋಜನೆಯ ವಿವಿಧ ಹಂತದ ಚಟುವಟಿಕೆಗಳು ಹಾಗೂ ಯೋಜನೆಗಳಿಂದ ಪ್ರಾರಂಭದ ಹಂತದ ತನಕ ವಿವಿಧ ಮೈಲುಗಲ್ಲುಗಳನ್ನು ತೋರಿಸುವ ಪರ್ಟ್ ನಕ್ಷೆಯನ್ನು ತಯಾರಿಸಿ ಮೇಲುಸ್ತುವಾರಿಗಾಗಿ ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತಕ್ಕೆ ಸಲ್ಲಿಸಬೇಕು.
6. ಎಲ್ಲೆಲ್ಲಿ ಶಾಸನಬದ್ಧ ಅನುಮೋದನೆ ಅವಶ್ಯಕತೆಯಿದೆಯೋ ಅಂದರೆ ಅರಣ್ಯ/ ಕಂದಾಯ/ ಪರಿಸರ ಮತ್ತು ಇತರ ಸಂಬಂಧಿತ ಇಲಾಖೆಗಳಿಂದ ಅನುಮೋದನೆಯನ್ನು ಹಂಚಿಕೆದಾರರು ಪಡೆದುಕೊಳ್ಳಬಹುದು.
7. ಮಂಡಳಿಯ ನೀತಿ ನಿಯಮಗಳಿಗನುಗುಣವಾಗಿ ಕರ್ನಾಟಕ ವಿದ್ಯುತ್ ಪ್ರಸರಣ ನಿಗಮ ನಿಯಮಿತಕ್ಕೆ ವೀಲಿಂಗ್ ಮತ್ತು ಬ್ಯಾಂಕಿಂಗ್/ ವಿದ್ಯುತ್ ಖರೀದಿ ಒಡಂಬಡಿಕೆ ಮಾಡಿಕೊಳ್ಳಲು ಅನುಮತಿಸಲಾಗಿದೆ.
8. ಕಾಲ ಕಾಲಕ್ಕೆ ಇರುವ ನೀತಿ ನಿಯಮಗಳಿಗೆ ಅನುಗುಣವಾಗಿ ಯಂತ್ರೋಪಕರಣಗಳಿಗೆ ಪ್ರವೇಶ ತೆರಿಗೆಯಿಂದ ವಿನಾಯಿತಿ ನೀಡಲಾಗಿದೆ.
9. ಯೋಜನೆಯನ್ನು ತ್ವರಿತವಾಗಿ ಮುಕ್ತಾಯ ಮಾಡಲು ಅನುವಾಗುವಂತೆ ರಾಜ್ಯ ಮತ್ತು ಜಿಲ್ಲಾ ಮಟ್ಟದ ಸರ್ಕಾರಿ ಅಧಿಕಾರಿಗಳು ಸಹಕರಿಸುವಂತೆ ವಿನಂತಿಸಲಾಗಿದೆ.
10. ಸದರಿ ಪವನ ವಿದ್ಯುತ್ ಯೋಜನೆಗಾಗಿ ಇಂಧನ ಇಲಾಖೆಯಿಂದ ಜಮೀನನ್ನು ಹಂಚಿಕೆ ಮಾಡಲಾಗುವುದಿಲ್ಲ ಹಾಗೂ ಈ ಹಂಚಿಕೆ ಆದೇಶವು ಅಭಿವೃದ್ಧಿದಾರರಿಗೆ ಯೋಜನೆಯ ಜಾಗದಲ್ಲಿಯ ಖನಿಜ ಸಂಪತ್ತು ಹಾಗೂ ಭೂಮಿಯ ಬಗ್ಗೆ ಯಾವುದೇ ಹಕ್ಕು ಇರುವುದಿಲ್ಲ ಎಂಬುದನ್ನು ಮನಗಾಣತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

**ಸುರೇಶ್ ಬಿ. ಕೃಷ್ಣಪ್ಪನವರ್**

ಪಿ.ಆರ್.1196

ಸರ್ಕಾರದ ಅಧೀನ ಕಾರ್ಯದರ್ಶಿ,
ಇಂಧನ ಇಲಾಖೆ.

## ಕಾನೂನು ಸಚಿವಾಲಯ

**ವಿಷಯ:** ಉಡುಪಿ ಜಿಲ್ಲೆಯ ನ್ಯಾಯಾಲಯಗಳನ್ನು ಖಾಯಂಗೊಳಿಸುವ ಬಗ್ಗೆ.

**ಓದಲಾಗಿದೆ:**
1) ಸರ್ಕಾರಿ ಆದೇಶ ಸಂಖ್ಯೆ: ಲಾ 183 ಎಲ್‌ಎಸಿ 1990, ದಿನಾಂಕ: 19.3.1992.
2) ಸರ್ಕಾರಿ ಆದೇಶ ಸಂಖ್ಯೆ: ಲಾ 185 ಎಲ್‌ಎಸಿ 95, ದಿನಾಂಕ: 29.3.1996.
3) ಸರ್ಕಾರಿ ಆದೇಶ ಸಂಖ್ಯೆ: ಲಾ 91 ಎಲ್‌ಎಸಿ 2005, ದಿನಾಂಕ: 19.4.2005.
4) ಪತ್ರ ಸಂಖ್ಯೆ: ಜಿಒಬಿ-2-93(14) 2005, ದಿನಾಂಕ: 24.3.2005.

**ಪ್ರಸ್ತಾವನೆ:**

ಉಡುಪಿ ಜಿಲ್ಲೆಯ ಈ ಕೆಳಗಿನ ನ್ಯಾಯಾಲಯಗಳನ್ನು ಕ್ರಮವಾಗಿ ಮೇಲೆ (1) ಮತ್ತು (2) ರಲ್ಲಿ ಓದಲಾದ ಆದೇಶಗಳಲ್ಲಿ ಸೃಜಿಸಲಾಗಿತ್ತು.

- 2ನೇ ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಕಿರಿಯ ವಿಭಾಗ) ಕಾರ್ಕಳ
- ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಹಿರಿಯ ವಿಭಾಗ) ಉಡುಪಿ

ನಂತರ ಸದರಿ ನ್ಯಾಯಾಲಯಗಳನ್ನು ಕಾಲಕಾಲಕ್ಕೆ ಮುಂದುವರೆಸಿಕೊಂಡು ಬರಲಾಗಿದ್ದು, ಇತ್ತೀಚೆಗೆ ಮೇಲೆ (3) ರಲ್ಲಿ ಓದಲಾದ ಆದೇಶದಲ್ಲಿ ದಿನಾಂಕ: 1.4.2005 ರಿಂದ ಒಂದು ವರ್ಷದ ಅವಧಿಗೆ ಮುಂದುವರಿಸಲಾಗಿತ್ತು.

ಈ ನ್ಯಾಯಾಲಯಗಳನ್ನು ಖಾಯಂಗೊಳಿಸುವಂತೆ ಮೇಲೆ (4) ರಲ್ಲಿ ಓದಲಾದ ಪತ್ರದಲ್ಲಿ ರಿಜಿಸ್ಟ್ರಾರ್ ಜನರಲ್, ಕರ್ನಾಟಕ ಉಚ್ಚ ನ್ಯಾಯಾಲಯ ಇವರು ಕೋರಿದ್ದಾರೆ.

ಪ್ರಸ್ತಾವನೆ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಲಾ 91 ಎಲ್‌ಎಸಿ 2005, ಬೆಂಗಳೂರು, ದಿನಾಂಕ: 23ನೇ ಆಗಸ್ಟ್ 2005**

ಉಡುಪಿ ಜಿಲ್ಲೆಯ ಈ ಕೆಳಗಿನ ನ್ಯಾಯಾಲಯಗಳನ್ನು ಅನುಬಂಧದಲ್ಲಿ ನಮೂದಿಸಿರುವ ಹುದ್ದೆಗಳ ಸಮೇತ ಈ ತಕ್ಷಣದಿಂದ ಜಾರಿಗೆ ಬರುವಂತೆ ಖಾಯಂಗೊಳಿಸಲು ಮಂಜೂರಾತಿ ನೀಡಲಾಗಿದೆ.

- 2ನೇ ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಕಿರಿಯ ವಿಭಾಗ) ಕಾರ್ಕಳ
- ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಹಿರಿಯ ವಿಭಾಗ) ಉಡುಪಿ

ಈ ನ್ಯಾಯಾಲಯಗಳ ವೆಚ್ಚವನ್ನು ಲೆಕ್ಕ ಶೀರ್ಷಿಕೆ “2014-00-105-0-01-ಯೋಜನೇತರ” ಅಡಿಯಲ್ಲಿ ಭರಿಸುವುದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 522 ವೆಚ್ಚ-7:05, ದಿನಾಂಕ: 12.7.2005 ರ ಸಹಮತಿಯ ಮೇರೆಗೆ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಎ.ಪಿ. ರಾಮಕೃಷ್ಣ**
ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),
ಕಾನೂನು ಇಲಾಖೆ (ಆಡಳಿತ-1).

**ಅನುಬಂಧ**

**ಸರ್ಕಾರಿ ಆದೇಶ ಸಂಖ್ಯೆ: ಲಾ 91 ಎಲ್‌ಎಸಿ 2005, ಬೆಂಗಳೂರು, ದಿನಾಂಕ: 23ನೇ ಆಗಸ್ಟ್ 2005**

| ಪದನಾಮ | 2ನೇ ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಕಿವಿ) ಕಾರ್ಕಳ | ಹೆಚ್ಚುವರಿ ಸಿವಿಲ್ ನ್ಯಾಯಾಧೀಶರು (ಹಿವಿ) ಉಡುಪಿ |
|---|---|---|
| 1) ಸಿವಿಲ್ ನ್ಯಾಯಾಧೀಶರು (ಕಿರಿಯ ವಿಭಾಗ) | 1 | - |
| 2) ಸಿವಿಲ್ ನ್ಯಾಯಾಧೀಶರು (ಹಿರಿಯ ವಿಭಾಗ) | - | 1 |
| 3) ಶೀಘ್ರಲಿಪಿಗಾರ | 1 | 1 |
| 4) ಪ್ರಥಮದರ್ಜೆ ಸಹಾಯಕ | 1 | 1 |
| 5) ಬೆರಳಚ್ಚುಗಾರ | 1 | 1 |
| 6) ಅಟೆಂಡರ್ | 1 | 1 |
| 7) ಪ್ಯೂನ್ | 2 | 2 |
| ಒಟ್ಟು | 7 | 7 |

**ಎ.ಪಿ. ರಾಮಕೃಷ್ಣ**
ಪಿ.ಆರ್.1211
ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),
ಕಾನೂನು ಇಲಾಖೆ (ಆಡಳಿತ-1).

**ವಿಷಯ:** ಗದಗ್ ಜಿಲ್ಲೆ ಮುಂಡರಗಿ ತಾಲ್ಲೂಕಿಗೆ ಹೆಚ್ಚುವರಿ ನೋಟರಿ ನೇಮಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂ: ಲಾ 13 ಎಲ್‌ಸಿಎಲ್ 04, ದಿನಾಂಕ: 29.1.05.
2) ಸರ್ಕಾರಿ ಪತ್ರ ಸಂಖ್ಯೆ: ಲಾ 93 ಎಲ್‌ಸಿಎಲ್ 05, ದಿನಾಂಕ: 5.4.05.
3) ಪತ್ರ 987/2005, ದಿನಾಂಕ: 2.6.2005.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ಸರ್ಕಾರಿ ಆದೇಶದಲ್ಲಿ ಗದಗ್ ಜಿಲ್ಲೆ ಮುಂಡರಗಿ ತಾಲ್ಲೂಕಿಗೆ ಒಂದು ನೋಟರಿ ಹುದ್ದೆಯನ್ನು ಹೆಚ್ಚುವರಿಯಾಗಿ ಸೃಜಿಸಲಾಗಿತ್ತು. ನಂತರ ಮೇಲೆ (2) ರಲ್ಲಿ ಓದಲಾದ ಸರ್ಕಾರಿ ಪತ್ರದಲ್ಲಿ ಸದರಿ ಹುದ್ದೆ ಭರ್ತಿ ಮಾಡಲು ಪ್ರಸ್ತಾವನೆ ಸಲ್ಲಿಸುವಂತೆ ಕೋರಲಾಗಿತ್ತು. ಆ ಮೇರೆಗೆ ಮೇಲೆ (3) ರಲ್ಲಿ ಓದಲಾದ ಪತ್ರದಲ್ಲಿ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಗದಗ್ ಇವರು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಸದರಿ ಪ್ರಸ್ತಾವನೆ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂಖ್ಯೆ: ಲಾ 93 ಎಲ್‌ಸಿಎಲ್ 2005, ಬೆಂಗಳೂರು, ದಿನಾಂಕ: 25ನೇ ಆಗಸ್ಟ್ 2005**

ನೋಟರಿ ನಿಯಮಾವಳಿಗಳ (1956) ನಿಯಮ 8(1)ರಲ್ಲಿ ಪ್ರದತ್ತವಾದ ಅಧಿಕಾರ ಚಲಾಯಿಸಿ ಶ್ರೀ ಬಸಪ್ಪ ಹನುಮಪ್ಪ ರಾಟಿ, ವಕೀಲರು, ಕೋಟೆಓಣಿ, ಮುಂಡರಗಿ, ಗದಗ್ ಜಿಲ್ಲೆ ಇವರನ್ನು ವೃತ್ತಿ ಪ್ರಮಾಣ ಪತ್ರ ನೀಡಲಾದ ದಿನಾಂಕದಿಂದ ಐದು ವರ್ಷಗಳ ಅವಧಿಗೆ ಮುಂಡರಗಿ ಕಂದಾಯ ತಾಲ್ಲೂಕಿಗೆ ನೋಟರಿಯನ್ನಾಗಿ ನೇಮಿಸಿದೆ.

ಸದರಿ ವಕೀಲರು “0070 ಇತರೆ ಆಡಳಿತಾತ್ಮಕ ಸೇವೆಗಳು-01 ನ್ಯಾಯ ಪರಿಪಾಲನೆ 501-0-ಇತರೆ ಸ್ವೀಕೃತಿಗಳು-06 ಇತರೆ ಬಾಬುಗಳು” ಈ ಲೆಕ್ಕ ಶೀರ್ಷಿಕೆಗೆ ಸರ್ಕಾರಿ ಖಜಾನೆಯಲ್ಲಿ ರೂ. 1000/- (ರೂಪಾಯಿ ಒಂದು ಸಾವಿರಗಳು ಮಾತ್ರ) ಶುಲ್ಕವನ್ನು ಜಮಾ ಮಾಡಿ ಆ ಬಗೆಗಿನ ಮೂಲ ಚಲನ್ ಮತ್ತು ಹುಟ್ಟಿದ ದಿನಾಂಕವನ್ನು ದೃಢೀಕರಿಸಬಲ್ಲ ದಾಖಲಾತಿ ಹಾಜರುಪಡಿಸಿದ ನಂತರ ಸದರಿಯವರಿಗೆ ವೃತ್ತಿ ಪ್ರಮಾಣ ಪತ್ರ ನೀಡಲಾಗುವುದು.

ತದನಂತರ ಶ್ರೀಯುತರ ಹೆಸರನ್ನು ನೋಟರಿ ಅಧಿನಿಯಮ 1952ರ ಕಲಂ 4ರ ಪ್ರಕಾರ ಸರ್ಕಾರ ನಿರ್ವಹಿಸುವ ರಿಜಿಸ್ಟರ್‌ನಲ್ಲಿ ನಮೂದಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
ಪಿ.ಆರ್. 1212
**ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**
ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),
ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಬಿಜಾಪುರ ಜಿಲ್ಲೆ, ಬಿಜಾಪುರ ಕಂದಾಯ ತಾಲ್ಲೂಕಿಗೆ ಎರಡು ನೋಟರಿ ಹುದ್ದೆಗಳನ್ನು ಹೆಚ್ಚುವರಿಯಾಗಿ ಸೃಜಿಸುವ ಬಗ್ಗೆ-ಆದೇಶ.

**ಪ್ರಸ್ತಾವನೆ:**

ಬಿಜಾಪುರ ಕಂದಾಯ ತಾಲ್ಲೂಕಿಗೆ ಆರು ಹುದ್ದೆಗಳನ್ನು ಈಗಾಗಲೇ ಮಂಜೂರು ಮಾಡಿದ್ದು ಮೂವರು ನೋಟರಿಗಳನ್ನು ಮಾತ್ರ ಕೆಲಸ ನಿರ್ವಹಿಸುತ್ತಿದ್ದಾರೆ. ಉಳಿದ ಮೂವರು ನೋಟರಿಗಳ ನವೀಕರಣಕ್ಕಾಗಿ 2001ನೇ ಸಾಲಿನಿಂದ ಬಾಕಿ ಇದ್ದು, ನ್ಯಾಯಾಲಯದಲ್ಲಿ W.P. (ರಿಟ್ ಪಿಟಿಷನ್‌ಗಳು) ದಾಖಲಾಗಿದೆ. ಈ ಬಗ್ಗೆ ನ್ಯಾಯಾಲಯದ ತೀರ್ಪು ಬಂದಿದ್ದರ ಹಿನ್ನೆಲೆಯಲ್ಲಿ ಸರ್ಕಾರದ ಪರಿಶೀಲನೆಯಲ್ಲಿದೆ. ಸದರಿ ತಾಲ್ಲೂಕಿನಲ್ಲಿ ಸದ್ಯಕ್ಕೆ ಮೂರು ನೋಟರಿಗಳು ಕರ್ತವ್ಯ ನಿರ್ವಹಿಸುತ್ತಿದ್ದು ಇವರಿಂದ ಸ್ಥಳೀಯವರ ಬೇಡಿಕೆಯನ್ನು ಪೂರೈಸಲು ಸಾಧ್ಯವಾಗುತ್ತಿಲ್ಲವಾದುದರಿಂದ ಈ ಹಿನ್ನೆಲೆಯನ್ನು ಗಮನಿಸಿ ಸರ್ಕಾರ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂ: ಲಾ 210 ಎಲ್‌ಸಿಎಲ್ 2005, ಬೆಂಗಳೂರು, ದಿನಾಂಕ: 24ನೇ ಆಗಸ್ಟ್ 2005**

ಮೇಲೆ ವಿವರಿಸಿರುವ ಅಂಶಗಳ ಹಿನ್ನಲೆಯಲ್ಲಿ ಬಿಜಾಪುರ ಕಂದಾಯ ತಾಲ್ಲೂಕಿಗೆ ಹೆಚ್ಚುವರಿಯಾಗಿ ಎರಡು ನೋಟರಿ ಹುದ್ದೆಗಳನ್ನು ಸೃಜಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1213 **ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**

ಸರ್ಕಾರದ ಅಧೀನ ಕಾರ್ಯದರ್ಶಿ,

ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಚಿತ್ರದುರ್ಗ ಜಿಲ್ಲೆ, ಹಿರಿಯೂರು ಕಂದಾಯ ತಾಲ್ಲೂಕು ಕ್ಷೇತ್ರಕ್ಕೆ ಒಂದು ನೋಟರಿ ಹುದ್ದೆಯನ್ನು ಹೆಚ್ಚುವರಿಯಾಗಿ ಸೃಜಿಸುವ ಬಗ್ಗೆ.

**ಓದಲಾಗಿದೆ:** 1) ದಿನಾಂಕ: 3.3.2004ರ ಅರಣ್ಯ ಸಚಿವರ ಆಪ್ತ ಕಾರ್ಯದರ್ಶಿ, ಇವರ ಟಿಪ್ಪಣಿ.

2) ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಚಿತ್ರದುರ್ಗ ಇವರ ಪತ್ರ ದಿನಾಂಕ: 7.5.2004.

**ಪ್ರಸ್ತಾವನೆ:**

ಮೇಲೆ ಓದಲಾಗಿರುವ ಕ್ರಮಾಂಕ (1) ದಿನಾಂಕ: 3.3.04ರ ಟಿಪ್ಪಣಿಯಲ್ಲಿ ಹಿರಿಯೂರು ಕ್ಷೇತ್ರದ ಜನಸಂಖ್ಯೆ ಹೆಚ್ಚಾಗಿರುವ ಹಿನ್ನಲೆಯಲ್ಲಿ ಹಿರಿಯೂರು ಕಂದಾಯ ತಾಲ್ಲೂಕಿಗೆ ಇನ್ನೊಂದು ನೋಟರಿ ಹುದ್ದೆ ಸೃಜಿಸುವಂತೆ ಕೋರಿರುತ್ತಾರೆ.

ಅದರಂತೆ ಈ ಬಗ್ಗೆ ಪರಿಶೀಲಿಸಲು ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು ಚಿತ್ರದುರ್ಗ ಇವರ ಅಭಿಪ್ರಾಯ ಕೋರಲಾಗಿ, ಮೇಲೆ ಓದಲಾದ ಕ್ರಮಾಂಕ (2)ರ ದಿನಾಂಕ: 7.5.2004ರ ಪತ್ರದಲ್ಲಿ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಚಿತ್ರದುರ್ಗ ಇವರು ಹಿರಿಯೂರು ತಾಲ್ಲೂಕಿನಲ್ಲಿ ಜನಸಂಖ್ಯೆ ಅಧಿಕವಾಗುತ್ತಿರುವ ಹಿನ್ನಲೆಯಲ್ಲಿ ಹೆಚ್ಚುವರಿಯಾಗಿ ಒಂದು ನೋಟರಿ ಹುದ್ದೆ ಸೃಜಿಸುವ ಅಗತ್ಯತೆ ಇದೆಯೆಂದು ಅಭಿಪ್ರಾಯ ನೀಡಿರುತ್ತಾರೆ. ಈ ಹಿನ್ನಲೆಯನ್ನು ಪರಿಗಣಿಸಿ ಸರ್ಕಾರವು ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂ: ಲಾ 30 ಎಲ್‌ಸಿಎಲ್ 2004, ಬೆಂಗಳೂರು, ದಿನಾಂಕ: 4ನೇ ಆಗಸ್ಟ್ 2005**

ಚಿತ್ರದುರ್ಗ ಜಿಲ್ಲೆಯ ಹಿರಿಯೂರು ಕಂದಾಯ ತಾಲ್ಲೂಕು ಕ್ಷೇತ್ರಕ್ಕೆ ಒಂದು ನೋಟರಿ ಹುದ್ದೆಯನ್ನು ಹೆಚ್ಚುವರಿಯಾಗಿ ಸೃಜಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1214 **ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),

ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಕೊಡಗು ಜಿಲ್ಲೆ ಸೋಮವಾರಪೇಟೆ ಕಂದಾಯ ತಾಲ್ಲೂಕಿಗೆ ನೋಟರಿ ನೇಮಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂ: ಲಾ 121 ಎಲ್‌ಸಿಎಲ್ 03, ದಿನಾಂಕ: 6.2.2004.

2) ಸರ್ಕಾರಿ ಸಮಸಂಖ್ಯೆ ಪತ್ರ: ದಿನಾಂಕ: 19.5.04.

3) ಪತ್ರ ಸಂಖ್ಯೆ: 2484/2004, ದಿನಾಂಕ: 7.7.04.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ಆದೇಶದಲ್ಲಿ ಸೋಮವಾರಪೇಟೆ ತಾಲ್ಲೂಕಿಗೆ ಒಂದು ನೋಟರಿ ಹುದ್ದೆಯನ್ನು ಹೆಚ್ಚುವರಿಯಾಗಿ ಸೃಜಿಸಲಾಗಿತ್ತು. ಸದರಿ ಹುದ್ದೆ ತುಂಬಲು ಪ್ರಸ್ತಾವನೆ ಸಲ್ಲಿಸುವಂತೆ ಮೇಲೆ (2) ರಲ್ಲಿ ಓದಲಾದ ಪತ್ರದಲ್ಲಿ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು ಕೊಡಗು ಇವರನ್ನು ಕೋರಲಾಗಿತ್ತು. ಆ ಮೇರೆಗೆ (3) ರಲ್ಲಿ ಓದಲಾದ ಪತ್ರದಲ್ಲಿ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ಕೊಡಗು ಇವರು ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಅದನ್ನು ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂ: ಲಾ 121 ಎಲ್‌ಸಿಎಲ್ 2003, ಬೆಂಗಳೂರು, ದಿನಾಂಕ: 25ನೇ ಆಗಸ್ಟ್ 2005**

ನೋಟರಿ ನಿಯಮಗಳ (1956) ನಿಯಮ 8(1) ರಲ್ಲಿ ಪ್ರದತ್ತವಾದ ಅಧಿಕಾರ ಚಲಾಯಿಸಿ ಶ್ರೀ ಹೆಚ್.ಬಿ. ಈಶ್ವರಚಂದ್ರ, ವಕೀಲರು, ದೇವಸ್ಥಾನದ ರಸ್ತೆ, ಸೋಮವಾರಪೇಟೆ, ಕೊಡಗು ಜಿಲ್ಲೆ ಇವರನ್ನು ವೃತ್ತಿ ಪ್ರಮಾಣ ಪತ್ರ ನೀಡಲಾದ ದಿನಾಂಕದಿಂದ ಐದು ವರ್ಷಗಳ ಅವಧಿಗೆ ಸೋಮವಾರಪೇಟೆ ಕಂದಾಯ ತಾಲ್ಲೂಕಿಗೆ ನೋಟರಿಯನ್ನಾಗಿ ನೇಮಿಸಿದೆ.

ಸದರಿ ವಕೀಲರು "0070 ಇತರೆ ಆಡಳಿತಾತ್ಮಕ ಸೇವೆಗಳು-01 ನ್ಯಾಯ ಪರಿಪಾಲನೆ 501-0-ಇತರೆ ಸ್ವೀಕೃತಿಗಳು-06 ಇತರೆ ಬಾಬುಗಳು" ಈ ಲೆಕ್ಕ ಶೀರ್ಷಿಕೆಗೆ ಸರ್ಕಾರಿ ಖಜಾನೆಯಲ್ಲಿ ನಿಗದಿಪಡಿಸಿದ ರೂ. 1000/- (ರೂಪಾಯಿ ಒಂದು ಸಾವಿರಗಳು ಮಾತ್ರ) ಶುಲ್ಕವನ್ನು ಜಮಾ ಮಾಡಿ ಈ ಬಗೆಗಿನ ಮೂಲ ಚಲನ್ ಮತ್ತು ಹುಟ್ಟಿದ ದಿನಾಂಕವನ್ನು ದೃಢೀಕರಿಸಬಲ್ಲ ದಾಖಲಾತಿ ಹಾಜರುಪಡಿಸಿದ ನಂತರ ಸದರಿಯವರಿಗೆ ವೃತ್ತಿ ಪ್ರಮಾಣ ಪತ್ರ ನೀಡಲಾಗುವುದು.

ತದನಂತರ ಶ್ರೀಯುತರ ಹೆಸರನ್ನು ನೋಟರಿ ಅಧಿನಿಯಮ 1952ರ ಕಲಂ 4ರ ಪ್ರಕಾರ ಸರ್ಕಾರ ನಿರ್ವಹಿಸುವ ರಿಜಿಸ್ಟರ್‌ನಲ್ಲಿ ನಮೂದಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1215

**ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),

ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಬಂಟ್ವಾಳ ಕಂದಾಯ ತಾಲ್ಲೂಕು (ದಕ್ಷಿಣ ಕನ್ನಡ ಜಿಲ್ಲೆ) ಇಲ್ಲಿಗೆ ನೋಟರಿ ನೇಮಿಸುವ ಬಗ್ಗೆ.

**ಓದಲಾಗಿದೆ:** 1) ಪತ್ರ ಸಂಖ್ಯೆ: ಲಾ 2 ಎಲ್‌ಸಿಎಲ್ 2005, ದಿನಾಂಕ: 5.4.2005.

2) ಪತ್ರ ಸಂ: ಎಡಿಎಂಎನ್: II/5557/2005, ದಿನಾಂಕ: 7.6.2005.

**ಪ್ರಸ್ತಾವನೆ:**

ಶ್ರೀ ಎಂ.ಎನ್. ರೈ, ನೋಟರಿ ಇವರ ನಿಧನದಿಂದ ತೆರವಾದ ನೋಟರಿ ಹುದ್ದೆ ತುಂಬಲು ಪ್ರಸ್ತಾವನೆ ಸಲ್ಲಿಸುವಂತೆ ಮೇಲೆ ಓದಲಾದ (1)ರ ಪತ್ರದಲ್ಲಿ ಕೋರಲಾಗಿತ್ತು. ಆ ಮೇರೆಗೆ, ಮೇಲೆ (2) ರಲ್ಲಿ ಓದಲಾಗಿರುವ ಪತ್ರದಲ್ಲಿ ಜಿಲ್ಲಾ ಮತ್ತು ಸತ್ರ ನ್ಯಾಯಾಧೀಶರು, ದಕ್ಷಿಣ ಕನ್ನಡ ಇವರು ಅರ್ಹ ಅಭ್ಯರ್ಥಿಗಳ ವಿವರಗಳನ್ನೊಳಗೊಂಡ ಪ್ರಸ್ತಾವನೆ ಸಲ್ಲಿಸಿರುತ್ತಾರೆ.

ಸದರಿ ಪ್ರಸ್ತಾವನೆ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರದ ಆದೇಶ ಸಂ: ಲಾ 02 ಎಲ್‌ಸಿಎಲ್ 2005, ಬೆಂಗಳೂರು, ದಿನಾಂಕ: 24ನೇ ಆಗಸ್ಟ್ 2005**

ನೋಟರಿ ನಿಯಮಗಳ (1956) ನಿಯಮ 8(1) ರಲ್ಲಿ ಪ್ರದತ್ತವಾದ ಅಧಿಕಾರ ಚಲಾಯಿಸಿ, ಶ್ರೀ ಅಶ್ವಿನಿ ಕುಮಾರ್ ರೈ ಎಂ. ವಕೀಲರು, ಬಿ.ಸಿ. ರಸ್ತೆ, ಜೋಡು ಮಾರ್ಗ, ಬಂಟ್ವಾಳ ತಾಲ್ಲೂಕು, ದಕ್ಷಿಣ ಕನ್ನಡ ಜಿಲ್ಲೆ, ಇವರನ್ನು (ವೃತ್ತಿ ಪ್ರಮಾಣ ಪತ್ರ ನೀಡಲಾದ ದಿನಾಂಕದಿಂದ) ಐದು ವರ್ಷಗಳ ಅವಧಿಗೆ ಬಂಟ್ವಾಳ ತಾಲ್ಲೂಕಿನ ನೋಟರಿಯನ್ನಾಗಿ ನೇಮಿಸಿದೆ.

ಸದರಿ ವಕೀಲರು ರೂ. 1000/- ಗಳ ಮೊತ್ತದ ಶುಲ್ಕವನ್ನು ಲೆಕ್ಕ ಶೀರ್ಷಿಕೆ "0070 ಇತರೆ ಆಡಳಿತಾತ್ಮಕ ಸೇವೆಗಳು-01 ನ್ಯಾಯ ಪರಿಪಾಲನೆ 501-0-ಇತರೆ ಸ್ವೀಕೃತಿಗಳು-06 ಇತರೆ ಬಾಬುಗಳು" ಗೆ ಪಾವತಿಸಿರುವ ಮೂಲ ಚಲನ್ ಸಲ್ಲಿಸುವುದರ ಜೊತೆಗೆ ಅವರ ಹುಟ್ಟಿದ ದಿನಾಂಕವನ್ನು ದೃಢೀಕರಿಸಬಲ್ಲ ದಾಖಲಾತಿ ಹಾಜರುಪಡಿಸಿದ ನಂತರ ವೃತ್ತಿ ಪ್ರಮಾಣ ಪತ್ರ ನೀಡಲಾಗುವುದು.

ತದನಂತರ ಶ್ರೀಯುತರ ಹೆಸರನ್ನು ನೋಟರಿ ಅಧಿನಿಯಮ (1952)ದ 4ನೇ ಪ್ರಕರಣದ ಪ್ರಕಾರ ಸರ್ಕಾರ ನಿರ್ವಹಿಸುತ್ತಿರುವ ರಿಜಿಸ್ಟರ್‌ನಲ್ಲಿ ನಮೂದಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1216

**ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),

ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಕೋಲಾರ ಜಿಲ್ಲೆ, ಗೌರಿಬಿದನೂರು, ಕಂದಾಯ ತಾಲ್ಲೂಕಿಗೆ ಹೆಚ್ಚುವರಿ ನೋಟರಿ ನೇಮಿಸುವ ಬಗ್ಗೆ.

**ಓದಲಾಗಿದೆ:** 1) ಸರ್ಕಾರಿ ಆದೇಶ ಸಂಖ್ಯೆ: ಲಾ 14 ಎಲ್‌ಸಿಎಲ್ 2000, ದಿನಾಂಕ: 21.5.01.

2) ರಿಟ್ ಅರ್ಜಿ ಸಂಖ್ಯೆ: 26913:2004- ಶ್ರೀ ಮುನಿಸ್ವಾಮಿ ರೆಡ್ಡಿ ಇವರು ರಾಜ್ಯ ಸರ್ಕಾರದ ವಿರುದ್ದ.

3) ಸರ್ಕಾರಿ ಪತ್ರ ಸಂ: ಲಾ 60 ಎಲ್‌ಡಬ್ಲ್ಯೂಪಿ 2004, ದಿನಾಂಕ: 4.2.2005.

**ಪ್ರಸ್ತಾವನೆ:**

ಶ್ರೀ ಮುನಿಸ್ವಾಮಿ ರೆಡ್ಡಿ, ನೋಟರಿ, ಗೌರಿಬಿದನೂರು, ಇವರು ನೋಟರಿ ಅಧಿನಿಯಮ (1952) ರ ಕಲಂ 9(1) ನ್ನು ಉಲ್ಲಂಘಿಸಿದ ಹಿನ್ನಲೆಯಲ್ಲಿ ಮೇಲೆ (1) ರಲ್ಲಿ ಓದಲಾದ ಆದೇಶದಲ್ಲಿ ಸದರಿಯವರನ್ನು ನೋಟರಿ ವೃತ್ತಿಯಿಂದ ತೆಗೆದುಹಾಕಲಾಗಿತ್ತು. ಸದರಿ ಆದೇಶವನ್ನು ಪ್ರಶ್ನಿಸಿ ಮೇಲೆ (2) ರಲ್ಲಿ ಓದಲಾದ ರಿಟ್ ಅರ್ಜಿಯನ್ನು ಉಚ್ಚ ನ್ಯಾಯಾಲಯದಲ್ಲಿ ಸಲ್ಲಿಸಿದ್ದರು.

ಈ ರಿಟ್ ಅರ್ಜಿಯಲ್ಲಿ ಉಚ್ಚ ನ್ಯಾಯಾಲಯವು ದಿನಾಂಕ: 6.9.2004 ರಂದು ತೀರ್ಪು ನೀಡುತ್ತಾ ಸದರಿಯವರ ಕೋರಿಕೆಯನ್ನು ಪುನಃ ಪರಿಶೀಲಿಸುವಂತೆ ಆದೇಶಿಸಿತ್ತು. ಈ ಪ್ರಕರಣದಲ್ಲಿ ಮೇಲ್ಮನವಿ ಸಲ್ಲಿಸದಿರಲು ಸರ್ಕಾರ ನಿರ್ಧರಿಸಿರುತ್ತದೆ.

ಈ ಹಿನ್ನಲೆಯಲ್ಲಿ ಪರಿಶೀಲಿಸಿ ಈ ಕೆಳಗಿನಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಲಾ 65 ಎಲ್‌ಸಿಎಲ್ 2004, ಬೆಂಗಳೂರು, ದಿನಾಂಕ: 17ನೇ ಆಗಸ್ಟ್ 2005**

ಕೋಲಾರ ಜಿಲ್ಲೆ, ಗೌರಿಬಿದನೂರು ಕಂದಾಯ ತಾಲ್ಲೂಕಿಗೆ ಒಂದು ಹೆಚ್ಚುವರಿ ನೋಟರಿ ಹುದ್ದೆಯನ್ನು ಸೃಜಿಸಿ ನೋಟರಿ ನಿಯಮಗಳ (1956) ನಿಯಮ 8(1) ರಲ್ಲಿ ಪ್ರದತ್ತವಾಗಿರುವ ಅಧಿಕಾರವನ್ನು ಚಲಾಯಿಸಿ ಶ್ರೀ ಮುನಿಸ್ವಾಮಿ ರೆಡ್ಡಿ, ವಕೀಲರು, ಗೌರಿಬಿದನೂರು, ಕೋಲಾರ ಜಿಲ್ಲೆ ಇವರಿಗೆ ವೃತ್ತಿ ಪ್ರಮಾಣ ಪತ್ರ ನೀಡುವ ದಿನಾಂಕದಿಂದ ಐದು ವರ್ಷಗಳ ಅವಧಿಗೆ ಹೊಸದಾಗಿ ಸೃಜಿಸಲಾದ ನೋಟರಿ ಹುದ್ದೆಗೆ ನೇಮಿಸಿ ಮುಂದುವರಿಸಲಾಗಿದೆ.

ಸದರಿ ವಕೀಲರು "ರೂ. 1,000/- (ರೂಪಾಯಿ ಒಂದು ಸಾವಿರಗಳು ಮಾತ್ರ) ಶುಲ್ಕವನ್ನು ಲೆಕ್ಕ ಶೀರ್ಷಿಕೆ "0070 ಇತರೆ ಆಡಳಿತಾತ್ಮಕ ಸೇವೆಗಳು-01 ನ್ಯಾಯ ಪರಿಪಾಲನೆ 501-0-ಇತರೆ ಸ್ವೀಕೃತಿಗಳು-06 ಇತರೆ ಬಾಬುಗಳು" ಜಮಾ ಮಾಡಿ ಆ ಬಗೆಗಿನ ಚಲನ್ ಜೊತೆಗೆ ಹುಟ್ಟಿದ ದಿನಾಂಕವನ್ನು ದೃಢೀಕರಿಸಬಲ್ಲ ದಾಖಲಾತಿ ಹಾಜರುಪಡಿಸಿದ ನಂತರ ವೃತ್ತಿ ಪ್ರಮಾಣ ಪತ್ರ ನೀಡಲಾಗುವುದು. ನಂತರ ನೋಟರಿ ಅಧಿನಿಯಮ (1952) ರ ಕಲಂ 4ರ ಪ್ರಕಾರ ಅವರ ಹೆಸರನ್ನು ಸರ್ಕಾರ ನಿರ್ವಹಿಸುವ ರಿಜಿಸ್ಟರ್‌ನಲ್ಲಿ ನಮೂದಿಸಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1217

**ಸಿ.ಎ. ಬಾಬು ರವೀಂದ್ರನಾಥ್ ಪಟೇಲ್**

ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),

ಕಾನೂನು ಇಲಾಖೆ (ಆಡಳಿತ-2).

**ವಿಷಯ:** ಶ್ರೀ ವಿ.ವೈ. ಕುಮಾರ್, ಅಪರ ಸರ್ಕಾರಿ ವಕೀಲರು, ಇವರ ವಿಮಾನ ಪ್ರಯಾಣ - ಘಟನೋತ್ತರ ಮಂಜೂರಾತಿ ಕುರಿತು.

**ಉಲ್ಲೇಖ:** ಅಡ್ವೋಕೇಟ್ ಜನರಲ್‌ರವರ ಅ.ಸ.ಪ. ಸಂ: 5:ಎಜಿಪಿ:2005-06, ದಿನಾಂಕ: 23.5.2005.

**ಸರ್ಕಾರದ ಆದೇಶ ಸಂ: ಲಾ 75 ಎಲ್‌ಎಜಿ 2005, ಬೆಂಗಳೂರು, ದಿನಾಂಕ: 18ನೇ ಆಗಸ್ಟ್ 2005**

ಶ್ರೀ ವಿ.ವೈ. ಕುಮಾರ್, ಅಪರ ಸರ್ಕಾರಿ ವಕೀಲರು, ಇವರು ಬೆಂಗಳೂರು ಮೈಸೂರು ನಡುವಿನ ಹೆದ್ದಾರಿ ಯೋಜನೆ ಕಾಮಗಾರಿ ಪ್ರಕರಣಕ್ಕೆ ಸಂಬಂಧಿಸಿದಂತೆ ಸರ್ವೋಚ್ಚ ನ್ಯಾಯಾಲಯದಲ್ಲಿ ಮೇಲ್ಮನವಿ ಸಲ್ಲಿಸಲು ದಿನಾಂಕ: 4.5.2005 ರಂದು ವಿಮಾನದ ಮೂಲಕ ಬೆಂಗಳೂರಿನಿಂದ ದೆಹಲಿಗೆ ಪ್ರಯಾಣಿಸಿ ದಿನಾಂಕ: 7.5.2005 ರಂದು ಹಿಂದಿರುಗಿರುವುದಕ್ಕೆ ಕರ್ನಾಟಕ ಕಾನೂನು ಅಧಿಕಾರಿಗಳ (ನೇಮಕಾತಿ ಮತ್ತು ಸೇವಾ ಸೌಲಭ್ಯಗಳು) ನಿಯಮಗಳು 1977ರ ನಿಯಮ 15 ರನ್ವಯ ಘಟನೋತ್ತರ ಮಂಜೂರಾತಿ ನೀಡಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1218

**ಎ.ಪಿ. ರಾಮಕೃಷ್ಣ**
ಸರ್ಕಾರದ ಅಧೀನ ಕಾರ್ಯದರ್ಶಿ (ಪ್ರಭಾರ),
ಕಾನೂನು ಇಲಾಖೆ (ಆಡಳಿತ-1).

## ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವಾಲಯ

**ವಿಷಯ:** ಡಾ: ಗಿರಿಜಾ ಸೂರಣಗಿ, ವೈದ್ಯರು ದರ್ಜೆ-2 ಸರ್ಕಾರಿ ಆಯುರ್ವೇದ ಆಸ್ಪತ್ರೆ ಚಿತ್ತಾಪುರ, ಗುಲ್ಬರ್ಗಾ ಜಿಲ್ಲೆ ಇವರ ವಿರುದ್ಧ ಶಿಸ್ತು ಕ್ರಮ ಜರುಗಿಸುವ ಬಗ್ಗೆ.

**ಉಲ್ಲೇಖ:**
1) ನಿರ್ದೇಶಕರು, ಭಾರತೀಯ ವೈದ್ಯಪದ್ಧತಿ ಮತ್ತು ಹೋಮಿಯೋಪತಿ ನಿರ್ದೇಶನಾಲಯ, ಇವರ ಪತ್ರ ಸಂಖ್ಯೆ: ಭಾವೈಪ. 97.ನಿ(4).2000-01, ದಿನಾಂಕ: 1.12.2003.
2) ಸರ್ಕಾರದ ಪತ್ರ ಸಂಖ್ಯೆ: ಆಕುಕ 680 ಪಿಐಎಂ 2002, ದಿನಾಂಕ: 17.12.2003.
3) ಸರ್ಕಾರದ ಪತ್ರ ಸಂಖ್ಯೆ: ಆಕುಕ 680 ಪಿಐಎಂ 2002, ದಿನಾಂಕ: 3.2.2004.
4) ಸರ್ಕಾರದ ಪತ್ರ ಸಂಖ್ಯೆ: ಆಕುಕ 680 ಪಿಐಎಂ 2002, ದಿನಾಂಕ: 16.2.2005.
5) ಕಾರ್ಯದರ್ಶಿ, ಕರ್ನಾಟಕ ಲೋಕಸೇವಾ ಆಯೋಗ, ಇವರ ಪತ್ರ ಸಂಖ್ಯೆ: ಪಿಎಸ್‌ಸಿ.153.ಸಿಎಸ್‌ಎನ್.2004, ದಿನಾಂಕ: 4.4.2005.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ನಿರ್ದೇಶಕರ ಪತ್ರದಲ್ಲಿ ಡಾ: ಗಿರಿಜಾ ಸೂರಣಗಿ, ವೈದ್ಯರು, ದರ್ಜೆ-2, ಸರ್ಕಾರಿ ಆಯುರ್ವೇದ ಚಿಕಿತ್ಸಾಲಯ, ಉತ್ತಂಗಿ, ಬಳ್ಳಾರಿ ಜಿಲ್ಲೆ ಇವರು ದಿನಾಂಕ: 1.1.2000 ರಿಂದ 31.12.2002 ರವರೆಗೆ ಕರ್ತವ್ಯಕ್ಕೆ ಅನಧಿಕೃತ ಗೈರು ಹಾಜರಾಗಿದ್ದು, ಸರ್ಕಾರದ ಅಧಿಸೂಚನೆ ಸಂಖ್ಯೆ: ಆಕುಕ 680 ಪಿಐಎಂ 2002, ದಿನಾಂಕ: 17.12.2002 ರನ್ವಯ ಸರ್ಕಾರಿ ಆಯುರ್ವೇದ ಆಸ್ಪತ್ರೆ, ಚಿತ್ತಾಪುರ ಇಲ್ಲಿ ಕರ್ತವ್ಯಕ್ಕೆ ವರದಿ ಮಾಡಿಕೊಂಡು ದಿನಾಂಕ: 6.6.2003 ರಿಂದ ಪುನಃ ಗೈರು ಹಾಜರಾಗಿರುವ ಬಗ್ಗೆ ಇಲಾಖಾ ವಿಚಾರಣೆ ನಡೆಸಲು ದೋಷಾರೋಪಣಾ ಪಟ್ಟಿಯನ್ನು ಅನುಬಂಧ-1 ರಿಂದ 4 ರವರೆಗೆ ಕಳುಹಿಸಿರುತ್ತಾರೆ.

ಮೇಲೆ (2) ರಲ್ಲಿ ಓದಲಾದ ಸರ್ಕಾರದ ಪತ್ರದಲ್ಲಿ ಡಾ: ಗಿರಿಜಾ ಸೂರಣಗಿ, ವೈದ್ಯರು, ದರ್ಜೆ-2, ಇವರ ವಿರುದ್ಧ ಕರ್ನಾಟಕ ನಾಗರೀಕ ಸೇವಾ (ವರ್ಗೀಕರಣ, ನಿಯಂತ್ರಣ ಮತ್ತು ಮೇಲ್ಮನವಿ) ನಿಯಮಗಳು 1957ರ ನಿಯಮ 11ರ ಪ್ರಕಾರ ಶಿಸ್ತು ಕ್ರಮ ಜರುಗಿಸಲು ನೋಟೀಸ್ ಜಾರಿ ಮಾಡಿ 15 ದಿನಗಳಲ್ಲಿ ರಕ್ಷಣಾ ಹೇಳಿಕೆಯನ್ನು ಲಿಖಿತ ಮೂಲಕ ಅಥವಾ ಮೌಖಿಕವಾಗಿ ತಿಳಿಸುವಂತೆ ಸೂಚಿಸಿ ರಕ್ಷಣಾ ಹೇಳಿಕೆಯನ್ನು ನಿಗದಿಪಡಿಸಿದ ಅವಧಿಯೊಳಗೆ ಸರ್ಕಾರಕ್ಕೆ ಸಲ್ಲಿಸದಿದ್ದಲ್ಲಿ ನಿಮ್ಮ ಹೇಳಿಕೆ ಏನು ಇಲ್ಲವೆಂದು ಭಾವಿಸಿ ಕರ್ನಾಟಕ ನಾಗರೀಕ ಸೇವಾ (ಸಿ.ಸಿ.ಎ.) ನಿಯಮಗಳು 1957ರ ಪ್ರಕಾರ ಕ್ರಮ ತೆಗೆದುಕೊಳ್ಳಲಾಗುವುದೆಂದು ಸೂಚಿಸಲಾಗಿದೆ.

ಡಾ: ಗಿರಿಜಾ ಸೂರಣಗಿ, ವೈದ್ಯರು, ದರ್ಜೆ-2, ಸರ್ಕಾರಿ ಆಯುರ್ವೇದ ಆಸ್ಪತ್ರೆ, ಚಿತ್ತಾಪುರ, ಗುಲ್ಬರ್ಗಾ ಜಿಲ್ಲೆ ಇವರಿಗೆ ಕಳುಹಿಸಲಾಗಿದ್ದ ಎಲ್ಲಾ ನೋಟೀಸ್‌ಗಳು ಜಾರಿಯಾಗದೇ ವಾಪಸ್ಸು ಬಂದಿದೆ. ಅವರು ಎಲ್ಲಿರುವರೆಂಬ ಬಗ್ಗೆ ವಿಳಾಸ ಗೊತ್ತಿಲ್ಲದ್ದರಿಂದ ಕೆ.ಸಿ.ಎಸ್. (ಸಿ.ಸಿ.ಎ) ನಿಯಮಾವಳಿಗಳು 1957ರ ನಿಯಮ 28(ಎ)(2) ರನ್ವಯ ಅಂತಿಮವಾಗಿ ರಾಜ್ಯಾದ್ಯಂತ ಅಧಿಕೃತವಾಗಿ ಪ್ರಚಲಿತವಿರುವ ಎರಡು ದಿನಪತ್ರಿಕೆಗಳಾದ ಪ್ರಜಾವಾಣಿ ಮತ್ತು ವಿಜಯ ಕರ್ನಾಟಕ ದಿನ ಪತ್ರಿಕೆಗಳಲ್ಲಿ ಪ್ರಕಟಿಸಿ 15 ದಿನಗಳೊಳಗಾಗಿ ರಕ್ಷಣಾ ಹೇಳಿಕೆಯನ್ನು ಸಲ್ಲಿಸುವಂತೆ ಇಲ್ಲದಿದ್ದಲ್ಲಿ ನಿಮ್ಮ ಹೇಳಿಕೆ ಏನು ಇಲ್ಲವೆಂದು ಭಾವಿಸಿ ನಿಯಮಾನುಸಾರ ಕ್ರಮ ತೆಗೆದುಕೊಳ್ಳಲಾಗುವುದೆಂದು ತಿಳಿಸಲಾಗಿತ್ತು. ಇದಕ್ಕೆ ಅವರಿಂದ ಉತ್ತರ ಬಂದಿರುವುದಿಲ್ಲ.

ಆದ್ದರಿಂದ ಅವರ ಹೇಳಿಕೆ ಏನೂ ಇಲ್ಲವೆಂದು ಪರಿಗಣಿಸಿ ಅನಧಿಕೃತ ಗೈರು ಹಾಜರಾಗಿರುವುದು ದೃಢಪಟ್ಟಿರುವ ನಿರ್ಣಯಕ್ಕೆ ಬರಲಾಗಿದ್ದು, ಸದರಿ ನಿಯಮಗಳ ನಿಯಮ 11ರ ಅಡಿಯಲ್ಲಿ ವಿಚಾರಣೆ ಮಾಡಲು ಸಾಧ್ಯವಾಗದೇ ಇರುವುದರಿಂದ ಹಾಗೂ ಸದರಿ ವೈದ್ಯರು ದಿನಾಂಕ: 29.2.2004 ರಂದು ಸೇವೆಯಿಂದ ವಯೋ ನಿವೃತ್ತಿ ಹೊಂದಿರುವುದರಿಂದ ಅವರನ್ನು ಸೇವೆಯಿಂದ ವಜಾಗೊಳಿಸುವ ದಂಡನೆಯನ್ನು ವಿಧಿಸಲು ನಿಯಮದಲ್ಲಿ ಅವಕಾಶವಿಲ್ಲದಿರುವುದರಿಂದ ಕರ್ನಾಟಕ ನಾಗರೀಕ ಸೇವಾ ನಿಯಮ 214ರ ಅಡಿಯಲ್ಲಿ ಇವರ ನಿವೃತ್ತಿ ವೇತನವನ್ನು ಸಂಪೂರ್ಣವಾಗಿ ಶಾಶ್ವತವಾಗಿ ತಡೆಹಿಡಿಯುವ ದಂಡನೆಯನ್ನು ವಿಧಿಸಲು ಹಾಗೂ ಸರ್ಕಾರಕ್ಕೆ ಇವರಿಂದ ಉಂಟಾಗಿರುವ ರೂ. 60,000.00 ಗಳ ಹಾನಿಯನ್ನು ಅವರ ನಿವೃತ್ತಿ ಸೌಲಭ್ಯದಿಂದ ಕಟಾಯಿಸಲು ಸರ್ಕಾರವು ತೀರ್ಮಾನಿಸಿ ಮೇಲೆ ಓದಲಾದ (4)ರ ಸರ್ಕಾರದ ಪತ್ರದಲ್ಲಿ ಕರ್ನಾಟಕ ಲೋಕಸೇವಾ ಆಯೋಗದ ಸಹಮತಿ ಕೋರಲಾಗಿತ್ತು. ಕರ್ನಾಟಕ ಲೋಕಸೇವಾ ಆಯೋಗವು ಮೇಲೆ ಓದಲಾದ (5)ರ ಪತ್ರದಲ್ಲಿ ವೈದ್ಯರ ನಿವೃತ್ತಿ ವೇತನವನ್ನು ಸಂಪೂರ್ಣವಾಗಿ ಮತ್ತು ಶಾಶ್ವತವಾಗಿ ತಡೆಹಿಡಿಯಲು ಹಾಗೂ ಅವರಿಂದ ಸರ್ಕಾರಕ್ಕೆ ಉಂಟಾಗಿರುವ ಹಾನಿ ರೂ. 60,000.00 ಗಳನ್ನು ಶೇ. 8 ರಂತೆ ಬಡ್ಡಿ ಸಮೇತ ಅವರ ನಿವೃತ್ತಿ ಸೌಲಭ್ಯದಿಂದ ಕಟಾಯಿಸುವುದು ಸೂಕ್ತವೆಂದು ಸಹಮತಿ ನೀಡಿದೆ. ಆದ್ದರಿಂದ ಈ ಆದೇಶ.

**ಸರ್ಕಾರದ ಆದೇಶ ಸಂಖ್ಯೆ: ಆಕುಕ 680 ಪಿಐಎಂ 2002, ಬೆಂಗಳೂರು, ದಿನಾಂಕ: 6ನೇ ಆಗಸ್ಟ್ 2005**

ಪ್ರಸ್ತಾವನೆಯಲ್ಲಿ ವಿವರಿಸಿರುವ ಕಾರಣಗಳಿಂದ ಡಾ: ಗಿರಿಜಾ ಸೂರಣಗಿ, ವೈದ್ಯರು, ದರ್ಜೆ-2 (ನಿವೃತ್ತಿ), ಸರ್ಕಾರಿ ಆಯುರ್ವೇದ ಆಸ್ಪತ್ರೆ, ಚಿತ್ತಾಪುರ, ಗುಲ್ಬರ್ಗಾ ಜಿಲ್ಲೆ ಇವರಿಗೆ ಕರ್ನಾಟಕ ನಾಗರೀಕ ಸೇವಾ ನಿಯಮಾವಳಿಗಳ ನಿಯಮ 214ರ ಅಡಿಯಲ್ಲಿ ಇವರ ನಿವೃತ್ತಿ ವೇತನವನ್ನು

ಸಂಪೂರ್ಣವಾಗಿ ಶಾಶ್ವತವಾಗಿ ತಡೆಹಿಡಿಯುವ ದಂಡನೆಯನ್ನು ಹಾಗೂ ಸರ್ಕಾರಕ್ಕೆ ಇವರಿಂದ ಉಂಟಾಗಿರುವ ರೂ. 60,000.00 (ಅರವತ್ತು ಸಾವಿರ ರೂಪಾಯಿಗಳು ಮಾತ್ರ) ಗಳ ಹಾನಿಯನ್ನು ಶೇ. 8 ರಂತೆ ಬಡ್ಡಿ ಸಮೇತ ಇವರ ನಿವೃತ್ತಿ ಸೌಲಭ್ಯದಿಂದ ಕಟಾಯಿಸಲು ಆದೇಶಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಎಸ್.ಕೆ. ತೆಗ್ಗಿನಮನಿ**

ಪಿ.ಆರ್.1234

ಸರ್ಕಾರದ ಅಧೀನ ಕಾರ್ಯದರ್ಶಿಗಳು,
ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ.

**ಆರ್ಥಿಕ ಸಚಿವಾಲಯ**

**ವಿಷಯ:** ಅಖಿಲ ಭಾರತ 72ನೇ ಕರ್ನಾಟಕ ಸಾಹಿತ್ಯ ಸಮ್ಮೇಳನದ ವೆಚ್ಚಕ್ಕಾಗಿ ಬೀದರ್ ಜಿಲ್ಲೆಯ ಸರ್ಕಾರಿ ನೌಕರರ ಒಂದು ದಿನದ ವೇತನವನ್ನು ವಂತಿಗೆಯಾಗಿ ನೀಡುವ ಬಗ್ಗೆ.

**ಓದಲಾಗಿದೆ:**
1. ಅಧ್ಯಕ್ಷರು, ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ ಜಿಲ್ಲಾ ಶಾಖೆ, ಬೀದರ್ ಇವರ ಪತ್ರ ಸಂಖ್ಯೆ:ಕರಸನೌಸಂಬಿ/2/2004–05 ದಿನಾಂಕ 12–4–2005.
2. ಅಧ್ಯಕ್ಷರು, ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಬೆಂಗಳೂರು ಇವರ ಪತ್ರ ಸಂಖ್ಯೆ:1257/2004–05 ದಿನಾಂಕ 13–4–2005.
3. ಅಧ್ಯಕ್ಷರು, ಕನ್ನಡ ಸಾಹಿತ್ಯ ಪರಿಷತ್ತು, ಬೆಂಗಳೂರು ಇವರು ಸರ್ಕಾರಕ್ಕೆ ಬರೆದಿರುವ ಪತ್ರ ದಿನಾಂಕ 31.5.2005.

**ಪ್ರಸ್ತಾವನೆ:**

ಮೇಲೆ (1) ರಲ್ಲಿ ಓದಲಾದ ದಿನಾಂಕ 12–4–2005ರ ಪತ್ರದಲ್ಲಿ, ಅಧ್ಯಕ್ಷರು, ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಬೀದರ್ ಶಾಖೆ, ಬೀದರ್ ಇವರು ಅಖಿಲ ಭಾರತ 72ನೇ ಕನ್ನಡ ಸಾಹಿತ್ಯ ಸಮ್ಮೇಳನವು ಬೀದರ್‌ನಲ್ಲಿ ಮೇ ತಿಂಗಳಲ್ಲಿ ಜರುಗಲಿದ್ದು, ಸದರಿ ಸಮ್ಮೇಳನದ ಖರ್ಚು ವೆಚ್ಚಕ್ಕಾಗಿ ಒಂದು ದಿನದ ವೇತನವನ್ನು ದೇಣಿಗೆಯಾಗಿ ನೀಡುವಂತೆ ಅಧ್ಯಕ್ಷರು, ಜಿಲ್ಲಾ ಕನ್ನಡ ಸಾಹಿತ್ಯ ಪರಿಷತ್ತು, ಬೀದರ್ ಇವರ ಕೋರಿಕೆಯ ಮೇರೆಗೆ, ದಿನಾಂಕ 29–3–2005 ಹಾಗೂ 11–4–2005 ರಂದು ನಡೆದ ಬೀದರ್ ಜಿಲ್ಲಾ ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘದ ಕಾರ್ಯಕಾರಿ ಸಮಿತಿ ಸಭೆಯಲ್ಲಿ ಸದರಿ ಸಾಹಿತ್ಯ ಸಮ್ಮೇಳನದ ವೆಚ್ಚವನ್ನು ಭರಿಸುವುದಕ್ಕಾಗಿ ಬೀದರ್ ಜಿಲ್ಲೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ರಾಜ್ಯ ಸರ್ಕಾರಿ ನೌಕರರ ಒಂದು ದಿನದ ವೇತನವನ್ನು ದೇಣಿಗೆಯಾಗಿ ನೀಡಲು ಸರ್ವಾನುಮತದ ನಿರ್ಣಯ ತೆಗೆದುಕೊಂಡಿದ್ದು, ಅದರಂತೆ, ದೇಣಿಗೆಯನ್ನು ಏಪ್ರಿಲ್ ಅಥವಾ ಮೇ ತಿಂಗಳ ವೇತನದಲ್ಲಿ ಕಟಾವುಗೊಳಿಸಿ ಅಖಿಲ ಭಾರತ 72ನೆಯ ಕನ್ನಡ ಸಾಹಿತ್ಯ ಸಮ್ಮೇಳನ ಸ್ವಾಗತ ಸಮಿತಿ, ಬೀದರ್ ಇವರ ನಿಧಿಗೆ ಜಮಾ ಮಾಡುವ ಕುರಿತು ಸರ್ಕಾರಿ ಆದೇಶ ಹೊರಡಿಸುವಂತೆ ಕೋರಿರುತ್ತಾರೆ. ಅಧ್ಯಕ್ಷರು, ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಬೆಂಗಳೂರು ಇವರೂ ಸಹ ಮೇಲೆ (2) ರಲ್ಲಿ ಓದಲಾದ 13–4–2005ರ ಪತ್ರದಲ್ಲಿ ಅಖಿಲ ಭಾರತ 72ನೇ ಕನ್ನಡ ಸಾಹಿತ್ಯ ಸಮ್ಮೇಳನದ ಖರ್ಚು ವೆಚ್ಚವನ್ನು ಭರಿಸುವುದಕ್ಕಾಗಿ ಬೀದರ್ ಜಿಲ್ಲಾ ಸರ್ಕಾರಿ ನೌಕರರು ಒಂದು ದಿನದ ವೇತನವನ್ನು ನೀಡಲು ಬೀದರ್ ಜಿಲ್ಲಾ ನೌಕರರ ಸಂಘವು ನಿರ್ಣಯ ತೆಗೆದುಕೊಂಡಿದ್ದು, ಅದರಂತೆ, ಏಪ್ರಿಲ್ ಅಥವಾ ಮೇ ತಿಂಗಳ ವೇತನದಲ್ಲಿ ಬೀದರ್ ಜಿಲ್ಲೆಯಲ್ಲಿ ಸೇವೆ ಸಲ್ಲಿಸುತ್ತಿರುವ ರಾಜ್ಯ ಸರ್ಕಾರಿ ನೌಕರರಿಂದ ಒಂದು ದಿನದ ವೇತನವನ್ನು ಕಟಾವುಗೊಳಿಸಿ ನಿಯಮಗಳನ್ವಯ ಸಾಹಿತ್ಯ ಸಮ್ಮೇಳನದ ಲೆಕ್ಕ ಶೀರ್ಷಿಕೆಗೆ ವರ್ಗಾಯಿಸಿ ಆದೇಶ ಹೊರಡಿಸುವಂತೆ ಕೋರಿರುತ್ತಾರೆ. ಮೇಲೆ (3) ರಲ್ಲಿ ಓದಲಾದ ದಿನಾಂಕ 31–5–2005ರ ಪತ್ರದಲ್ಲಿ ಅಧ್ಯಕ್ಷರು, ಕನ್ನಡ ಸಾಹಿತ್ಯ ಪರಿಷತ್ತು, ಬೆಂಗಳೂರು ಇವರು ಅಖಿಲ ಭಾರತ 72ನೇ ಕನ್ನಡ ಸಾಹಿತ್ಯ ಸಮ್ಮೇಳನವು ಬೀದರ್‌ನಲ್ಲಿ **ನವೆಂಬರ್ ತಿಂಗಳ 18, 19, 20 ರಂದು** 3 ದಿನಗಳ ಕಾಲ ನಡೆಯಲಿದ್ದು, ಸದರಿ ಸಮ್ಮೇಳನಕ್ಕೆ ಬೀದರ್ ಜಿಲ್ಲೆಯ ಸರ್ಕಾರಿ ನೌಕರರು/ಅರೆ ಸರ್ಕಾರಿ ನೌಕರರು ಒಂದು ದಿನದ ವೇತನವನ್ನು ಕೊಡುಗೆಯಾಗಿ ನೀಡಲು ಈಗಾಗಲೇ ಒಪ್ಪಿದ್ದು, ಆಗಸ್ಟ್/ಸೆಪ್ಟೆಂಬರ್ ತಿಂಗಳ ಸಂಬಳದಲ್ಲಿ ಈ ಕೊಡುಗೆಯನ್ನು ಕಡಿತಗೊಳಿಸಲು ಸೂಕ್ತ ಆದೇಶ ಹೊರಡಿಸುವಂತೆ ಕೋರಿರುತ್ತಾರೆ.

ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಜಿಲ್ಲಾ ಶಾಖೆ, ಬೀದರ್ ಹಾಗೂ ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಬೆಂಗಳೂರು ಇವರ ಕೋರಿಕೆಯನ್ನು ಕೂಲಂಕಷವಾಗಿ ಪರಿಶೀಲಿಸಿ ಸರ್ಕಾರವು ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಆಇ 28 ಎಸ್‌ಆರ್‌ಪಿ 2005, ಬೆಂಗಳೂರು, ದಿನಾಂಕ: 11ನೇ ಆಗಸ್ಟ್ 2005.**

ಪ್ರಸ್ತಾವನೆಯಲ್ಲಿ ವಿವರಿಸಿದ ಕಾರಣಗಳ ಹಿನ್ನೆಲೆಯಲ್ಲಿ, ಪ್ರಸ್ತಾವಿತ ಅಖಿಲ ಭಾರತ 72ನೇ ಕನ್ನಡ ಸಾಹಿತ್ಯ ಸಮ್ಮೇಳನವು **ನವೆಂಬರ್ 2005ರ 18, 19, 20 ರಂದು** ಬೀದರ್‌ನಲ್ಲಿ ನಡೆಯಲಿದ್ದು, ಸದರಿ ಸಮ್ಮೇಳನದ ಖರ್ಚು ವೆಚ್ಚಗಳನ್ನು ಭರಿಸುವ ಸಲುವಾಗಿ ಬೀದರ್ ಜಿಲ್ಲೆಯ ಸರ್ಕಾರಿ ನೌಕರರು ಒಂದು ದಿನದ ವೇತನವನ್ನು ವಂತಿಕೆ ರೂಪದಲ್ಲಿ ನೀಡಲು, ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘ, ಜಿಲ್ಲಾ ಶಾಖೆ, ಬೀದರ್ ಇವರು ದಿನಾಂಕ 29–3–2005 ಮತ್ತು 11–4–2005 ರಂದು ಜರುಗಿದ ಕಾರ್ಯಕಾರಿ ಸಮಿತಿ ಸಭೆಯಲ್ಲಿ ತೆಗೆದುಕೊಂಡಿರುವ ತೀರ್ಮಾನವನ್ನು ಹಾಗೂ ಕರ್ನಾಟಕ ರಾಜ್ಯ ಸರ್ಕಾರಿ ನೌಕರರ ಸಂಘದ ಅಧ್ಯಕ್ಷರು, ಈ ಕುರಿತು ದಿನಾಂಕ:13–4–2005 ರ ತಮ್ಮ ಪತ್ರದಲ್ಲಿ ಮಾಡಿರುವ ಮನವಿಯನ್ನು ಪರಿಗಣಿಸಿ, ಬೀದರ್ ಜಿಲ್ಲೆಯಲ್ಲಿ ಕೆಲಸ ನಿರ್ವಹಿಸುತ್ತಿರುವ ರಾಜ್ಯ ಸರ್ಕಾರಿ ನೌಕರರ ಒಂದು ದಿನದ ವೇತನವನ್ನು ಸೆಪ್ಟೆಂಬರ್ 2005ರ ಮಾಹೆಯ ವೇತನದಲ್ಲಿ ಕಟಾಯಿಸಲು ಸರ್ಕಾರವು ಮಂಜೂರಾತಿ ನೀಡಿದೆ. ಹೀಗೆ ಕಟಾಯಿಸಿದ ಒಟ್ಟು ಮೊತ್ತಕ್ಕೆ ಜಿಲ್ಲಾಧಿಕಾರಿಗಳು, ಬೀದರ್ ಜಿಲ್ಲೆ, ಬೀದರ್ ಇವರಿಗೆ ಕ್ರೋಢೀಕೃತ ಚೆಕ್ಕನ್ನು ನೀಡುವುದು ಹಾಗೂ ಈ ಕುರಿತು ಹಣ ಸಂದಾಯ ಮಾಡುವ ವಿಧಿ ವಿಧಾನಗಳು ಈ ಕೆಳಗಿನಂತಿದೆ:–

ಅ) ನೌಕರರ ಒಂದು ದಿನದ ವೇತನ ವಂತಿಗೆಯನ್ನು 2005ರ ಸೆಪ್ಟೆಂಬರ್ ತಿಂಗಳ ವೇತನದ ಬಿಲ್ಲಿನಿಂದ ಕಟಾವುಗೊಳಿಸುವ ಮೂಲಕ ವಸೂಲು ಮಾಡಲು ಆಯಾ ಕಛೇರಿ ಮುಖ್ಯಾಧಿಕಾರಿಗಳು ಮತ್ತು ಖಜಾನಾಧಿಕಾರಿಗಳು ಅಧಿಕಾರ ಪಡೆದಿರುತ್ತಾರೆ.

ಆ) ಒಂದು ದಿನದ ವೇತನವನ್ನು ವಂತಿಗೆಯಾಗಿ ಕೊಡಲಿಚ್ಛಿಸದ ನೌಕರರು ತಮ್ಮ ಅಸಮ್ಮತಿಯನ್ನು ಸಂಬಂಧಪಟ್ಟ ಬಟವಾಡೆ ಅಧಿಕಾರಿಗಳಿಗೆ ಲಿಖಿತ ಮೂಲಕ ಸಲ್ಲಿಸತಕ್ಕದ್ದು ಮತ್ತು ಅಂತಹ ಲಿಖಿತ ಪತ್ರ ನೌಕರರಿಂದ ಸೆಪ್ಟೆಂಬರ್ ತಿಂಗಳಿನ ಸಂಬಳದ ಬಿಲ್ಲನ್ನು ಖಜಾನೆಗೆ ಸಲ್ಲಿಸುವ ದಿನಾಂಕದ ಒಳಗಾಗಿ ಬಂದಿದ್ದಲ್ಲಿ ಮಾತ್ರ ಅಂತಹ ನೌಕರನ/ಳ ಒಂದು ದಿನದ ವೇತನವನ್ನು 2005ರ ಸೆಪ್ಟೆಂಬರ್ ತಿಂಗಳಿನ ವೇತನ ಬಿಲ್ಲಿನಲ್ಲಿ ಕಟಾವು ಮಾಡತಕ್ಕದ್ದಲ್ಲ.

ಇ) ಪ್ರತಿಯೊಬ್ಬ ನೌಕರನ/ಳ ಕಟಾಯಿಸಿದ ಒಂದು ದಿನದ ವೇತನದ ಮೊತ್ತವನ್ನು ಬಿಲ್ಲಿನಲ್ಲಿ ಅವರ ಹೆಸರಿನ ಎದುರಿನಲ್ಲಿ **"72ನೇ ಅಖಿಲ ಭಾರತ ಕನ್ನಡ ಸಾಹಿತ್ಯ ಸಮ್ಮೇಳನಕ್ಕಾಗಿ ವಂತಿಕೆ"** ಎಂದು ಪ್ರತ್ಯೇಕ ಅಂಕಣದಲ್ಲಿ ಕಾಣಿಸಬೇಕು ಮತ್ತು ಸಮಗ್ರ ವೇತನ ವೇತನ ಬಿಲ್ಲಿನಲ್ಲಿ ಕಡಿತಗೊಳಿಸಿದ ಒಟ್ಟು ಮೊತ್ತವನ್ನು ವೇತನ ಬಿಲ್ಲಿನ ಮುಖ ಪುಟದಲ್ಲಿ **"72ನೇ ಅಖಿಲ ಭಾರತ ಕನ್ನಡ ಸಾಹಿತ್ಯ ಸಮ್ಮೇಳನಕ್ಕಾಗಿ ವಂತಿಕೆ"** ಎಂಬುದಾಗಿ ಸ್ಪಷ್ಟವಾಗಿ ನಮೂದಿಸಬೇಕು. ಜಿಲ್ಲಾ ಖಜಾನೆ ಅಧಿಕಾರಿಗಳು ಒಟ್ಟು ಮೊತ್ತವನ್ನು ಈ ಕೆಳಗೆ ನಮೂದಿಸಿರುವ ಲೆಕ್ಕ ಶೀರ್ಷಿಕೆಗೆ ವರ್ಗಾವಣೆ ಜಮಾ ಮೂಲಕ ಬಿಲ್ಲನ್ನು ಪಾವತಿ ಮಾಡಬೇಕು. ವೇತನ ಬಟವಾಡೆ ಮಾಡಲು ನಿವ್ವಳ ಮೊತ್ತಕ್ಕೆ ಚೆಕ್ಕನ್ನು ಬಟವಾಡೆ ಅಧಿಕಾರಿಗೆ ಅವರು ನೀಡಬೇಕು.

ಈ) 72ನೇ ಅಖಿಲ ಭಾರತ ಕನ್ನಡ ಸಾಹಿತ್ಯ ಸಮ್ಮೇಳನಕ್ಕಾಗಿ ಬೀದರ್ ಜಿಲ್ಲೆಯ ರಾಜ್ಯ ಸರ್ಕಾರಿ ಅಧಿಕಾರಿ/ನೌಕರರ ಒಂದು ದಿನದ ವೇತನ ಕಟಾಯಿಸುವುದನ್ನು, ಲೆಕ್ಕಶೀರ್ಷಿಕೆ **"8658-00-102-4-16, ವಂತಿಕೆಗಳು–72ನೇ ಕನ್ನಡ ಸಾಹಿತ್ಯ ಸಮ್ಮೇಳನ, ಬೀದರ್"** ರಡಿ ಜಮಾ ಮಾಡತಕ್ಕದ್ದು. ಹೀಗೆ ಜಮಾ ಮಾಡುವ ಒಟ್ಟು ಮೊತ್ತಕ್ಕೆ ಜಿಲ್ಲಾ ಖಜಾನೆ ಅಧಿಕಾರಿಯು ಜಿಲ್ಲಾಧಿಕಾರಿಗಳು, ಬೀದರ್ ಜಿಲ್ಲೆ, ಬೀದರ್ ಇವರಿಗೆ ಕ್ರೋಢೀಕೃತ ಮೊಬಲಗಿಗೆ ಚೆಕ್ಕನ್ನು ನೀಡುವುದು.

ಉ) 2005ರ ಸೆಪ್ಟೆಂಬರ್ ತಿಂಗಳಿನಲ್ಲಿ ಸ್ವೀಕರಿಸಲಾದ ವೇತನ ಬಿಲ್ಲುಗಳ ನಿರ್ವಹಣೆಯನ್ನು 2005ರ ಅಕ್ಟೋಬರ್ 10ನೇ ದಿನಾಂಕದೊಳಗೆ ಪೂರೈಸಬೇಕು. ಸೆಪ್ಟೆಂಬರ್ ತಿಂಗಳು ಅಂತ್ಯಗೊಂಡ ನಂತರ ಪಾವತಿ ಮಾಡಿದ ಬಿಲ್ಲುಗಳ ಪ್ರಕರಣಗಳಲ್ಲಿ ಅವುಗಳನ್ನು ಪಾವತಿ ಮಾಡಿದ ಒಂದು ವಾರದೊಳಗೆ ಜಿಲ್ಲಾಧಿಕಾರಿಗಳು, ಬೀದರ್ ಜಿಲ್ಲೆ, ಬೀದರ್ ಇವರಿಗೆ ಚೆಕ್ಕನ್ನು ಕಳುಹಿಸಬೇಕು ಹಾಗೂ ಹೀಗೆ ಕೈಗೊಂಡ ಕ್ರಮದ ಬಗ್ಗೆ ಒಂದು ಪ್ರತಿಯನ್ನು ಆರ್ಥಿಕ ಇಲಾಖೆಗೆ ಕಳುಹಿಸಬೇಕು.

ಊ) ಮಹಾಲೇಖಪಾಲರು ನೀಡಿದ ಅಧಿಕಾರ ಪತ್ರದ ಮೇಲೆ ತಮ್ಮ ವೇತನವನ್ನು ಖಜಾನೆಯಿಂದ ಪಡೆಯುವ ಅಧಿಕಾರಿಗಳೂ ಸಹ ಮೇಲೆ ಕಾಣಿಸಿದ ಕ್ರಮವನ್ನು ಪಾಲಿಸುವುದು.

ಋ) ಜಿಲ್ಲಾಧಿಕಾರಿ, ಬೀದರ್ ಜಿಲ್ಲೆ ಅವರು ಈ ವಂತಿಕೆ ಹಣವನ್ನು ಉದ್ದೇಶಿತ ಯೋಜನೆಗೆ ಬಳಸಿಕೊಳ್ಳಲು ಅಧಿಕಾರ ಹೊಂದಿರುತ್ತಾರೆ.

ಕರ್ನಾಟಕ ರಾಜ್ಯಪಾಲರ ಆದೇಶಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1235

**ಎನ್.ಟಿ.ನಾಯ್ಕ್**
ಸರ್ಕಾರದ ಉಪ ಕಾರ್ಯದರ್ಶಿ,
ಆರ್ಥಿಕ ಇಲಾಖೆ (ಸೇವೆಗಳು–2).

## ಜಲಸಂಪನ್ಮೂಲ ಸಚಿವಾಲಯ

**ವಿಷಯ:** ಗುಲ್ಬರ್ಗಾ ಜಿಲ್ಲೆ, ಆಳಂದ ತಾಲ್ಲೂಕು ಸಾಲೆಗಾಂವ ಗ್ರಾಮದ ಸಾಲೆಗಾಂವ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಭೂಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ನ್ಯಾಯಾಲಯದ ಆದೇಶದಂತೆ ಹೆಚ್ಚಿನ ಪರಿಹಾರಧನ ಪಾವತಿಸುವ ಕುರಿತು.

**ಓದಲಾಗಿದೆ:** ಕಾರ್ಯನಿರ್ವಾಹಕ ಇಂಜಿನಿಯರ್ ಸಣ್ಣ ನೀರಾವರಿ ವಿಭಾಗ, ಗುಲ್ಬರ್ಗಾ ಇವರ ದಿನಾಂಕ: 17.3.2005ರ ಪತ್ರ ಸಂ: ಸನೀವಿಗು/ಭೂಸ್ವಾ/2005-06.

**ಪ್ರಸ್ತಾವನೆ:**

ಮೇಲೆ ಓದಲಾದ ದಿನಾಂಕ: 17.3.2005ರ ಪತ್ರದಲ್ಲಿ ಕಾರ್ಯನಿರ್ವಾಹಕ ಇಂಜಿನಿಯರ್ ಸಣ್ಣ ನೀರಾವರಿ ವಿಭಾಗ, ಗುಲ್ಬರ್ಗಾ ಇವರು ಗುಲ್ಬರ್ಗಾ ಜಿಲ್ಲೆ, ಆಳಂದ ತಾಲ್ಲೂಕು ಸಾಲೆಗಾಂವ ಗ್ರಾಮದ ಸಾಲೆಗಾಂವ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಭೂಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಗುಲ್ಬರ್ಗಾದ ಮಾನ್ಯ ಹೆಚ್ಚುವರಿ ಸಿವಿಲ್ ನ್ಯಾಯಾಲಯದ (ಹಿರಿಯ ಶ್ರೇಣಿ) ಆದೇಶಾನುಸಾರ ಹೆಚ್ಚಿನ ಪರಿಹಾರಧನ ಪಾವತಿಸಲು ರೂ. 30,889.00 ಗಳ ಅನುದಾನ ಬಿಡುಗಡೆ ಮಾಡುವಂತೆ ಕೋರಿದ್ದಾರೆ. ಈ ಪ್ರಕರಣದ ವಿವರಗಳು ಈ ಕೆಳಕಂಡಂತಿವೆ:

- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 4(1) ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 14.6.1990.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯ ಕಲಂ 6(1)ರಡಿ ಅಧಿಸೂಚನೆ ಹೊರಡಿಸಿದ ದಿನಾಂಕ: 20.6.1991.
- ಕರ್ನಾಟಕ ಭೂಸ್ವಾಧೀನ ಕಾಯ್ದೆಯಡಿಯಲ್ಲಿ ಅವಾರ್ಡ್ ಘೋಷಿಸಿದ ದಿನಾಂಕ: 25.5.1993.
- ಜಮೀನಿನ ಕಬ್ಜ ಪಡೆದ ದಿನಾಂಕ: 20.1.1973.

ಐತೀರ್ಪಿನಂತೆ ಪರಿಹಾರಧನ ಪಡೆದ ಭೂಮಾಲೀಕರು ಹೆಚ್ಚಿನ ಪರಿಹಾರಧನಕ್ಕಾಗಿ ಭೂಸ್ವಾಧೀನ ಕಾಯ್ದೆ 18(1) ರನ್ವಯ ಗುಲ್ಬರ್ಗಾದ ಹೆಚ್ಚುವರಿ ಸಿವಿಲ್ ನ್ಯಾಯಾಲಯ (ಹಿರಿಯ ಶ್ರೇಣಿ) ದಲ್ಲಿ ಭೂಸ್ವಾಧೀನ ಪ್ರಕರಣಗಳನ್ನು ದಾಖಲಿಸಿ ಮಾನ್ಯ ನ್ಯಾಯಾಲಯದಿಂದ ಹೆಚ್ಚಿನ ಪರಿಹಾರಕ್ಕೆ ಆದೇಶ ಪಡೆದುಕೊಂಡಿದ್ದಾರೆ.

| ಕ್ರ.ಸಂ. | ಎಲ್.ಎ.ಸಿ. ಪ್ರಕರಣ ಸಂ. | ನ್ಯಾಯಾಲಯದ ಆದೇಶದ ದಿನಾಂಕ | ಸ.ನಂ. | ವಿಸ್ತೀರ್ಣ ಎ-ಗುಂ. | ಪರಿಹಾರ ಮೊತ್ತ ರೂ.ಗಳಲ್ಲಿ (ಬಡ್ಡಿ ಎಲ್ಲಾ ಅಂಶಗಳು ಸೇರಿ ಲೆಕ್ಕಾಚಾರ ತಃಖ್ತೆಯಂತೆ) |
|---|---|---|---|---|---|
| 1 | 17/97 | 15.3.2000 | 99/2 | 0-06 | 1898.00 |
| 2 | 18/97 | 15.3.2000 | 8/6 | 0-01 | 10896.00 |
| 3 | 19/97 | 15.3.2000 | 9/4 | 0-10 | 18095.00 |
| | | | | ಒಟ್ಟು | 30889.00 |

ಮೇಲ್ಕಂಡ ಎಲ್.ಎ.ಸಿ. ಪ್ರಕರಣಗಳಲ್ಲಿ ಆಗಿದ್ದ ಆದೇಶಗಳ ಬಗ್ಗೆ ಕಾನೂನು ಇಲಾಖೆ ತಮ್ಮ ಪತ್ರ ಸಂ: ಲಾ/421-ಎಲ್ಎಸ್‌ಜಿ 2000 ದಿನಾಂಕ: 4.7.2000 ರಂತೆ ಈ ಆದೇಶಗಳ ವಿರುದ್ಧ ಮೇಲ್ಮನವಿ ಸಲ್ಲಿಸದಿರಲು ತೀರ್ಮಾನಿಸಿದೆ.

ಪ್ರಸ್ತಾವನೆಯನ್ನು ಸರ್ಕಾರದ ಮಟ್ಟದಲ್ಲಿ ಕೂಲಂಕುಷವಾಗಿ ಪರಿಶೀಲಿಸಿ ಈ ಕೆಳಕಂಡಂತೆ ಆದೇಶ ಹೊರಡಿಸಲಾಗಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸನೀಇ 59 ಭೂಸ್ವಾಪ್ರ 2005, ಬೆಂಗಳೂರು, ದಿನಾಂಕ: 1ನೇ ಸೆಪ್ಟೆಂಬರ್ 2005**

ಗುಲ್ಬರ್ಗಾ ಜಿಲ್ಲೆ ಆಳಂದ ತಾಲ್ಲೂಕು ಸಾಲೆಗಾಂವ ಗ್ರಾಮದ ಸಾಲೆಗಾಂವ ಸಣ್ಣ ನೀರಾವರಿ ಕೆರೆ ನಿರ್ಮಾಣಕ್ಕಾಗಿ ಸ್ವಾಧೀನಪಡಿಸಿಕೊಳ್ಳಲಾದ ಜಮೀನುಗಳಿಗೆ ಗುಲ್ಬರ್ಗಾದ ಸಿವಿಲ್ ನ್ಯಾಯಾಲಯ (ಹಿರಿಯ ಶ್ರೇಣಿ) ದ ಆದೇಶದನ್ವಯ ಪರಿಹಾರಧನ ರೂ. 30,889.00 (ಮೂವತ್ತು ಸಾವಿರದ ಎಂಟುನೂರ ಎಂಭತ್ತೊಂಭತ್ತು ರೂಪಾಯಿಗಳು ಮಾತ್ರ) ಗಳನ್ನು ಪ್ರಸ್ತಾವನೆಯಲ್ಲಿ ವಿವರಿಸಿರುವಂತೆ ಪಾವತಿಸಲು ಸರ್ಕಾರವು ಅನುಮೋದನೆ ನೀಡಿದೆ. ಪಾವತಿಸುವ ಮುನ್ನ ಮತ್ತೊಮ್ಮೆ ಲೆಕ್ಕಾಚಾರ ತಃಖ್ತೆಯನ್ನು ದೃಢೀಕರಿಸಿಕೊಂಡು ಸರ್ಕಾರಕ್ಕೆ ಅಧಿಕ ಆರ್ಥಿಕ ವೆಚ್ಚವಾಗದಂತೆ ಪಾವತಿಸುವುದು.

ಈ ವೆಚ್ಚವನ್ನು 2005-06ನೇ ಸಾಲಿನ ಆಯವ್ಯಯದ ಲೆಕ್ಕಶೀರ್ಷಿಕೆ 4702-00-800-1-00-ಭೂಸ್ವಾಧೀನ ವೆಚ್ಚಗಳು ಮತ್ತು ಕ್ಲೇಮುಗಳು-ಇತ್ಯರ್ಥ 132 ಬಂಡವಾಳ ವೆಚ್ಚಗಳು ಅಡಿಯಲ್ಲಿ ಸಣ್ಣ ನೀರಾವರಿ ಇಲಾಖೆಗೆ ಒದಗಿಸಿರುವ ಅನುದಾನದಿಂದ ಭರಿಸಿಕೊಳ್ಳತಕ್ಕದ್ದು.

ಈ ಆದೇಶವನ್ನು ಆರ್ಥಿಕ ಇಲಾಖೆಯ ಆದೇಶ ಸಂ: ಎಫ್‌ಡಿ 1 ಟಿಎಫ್‌ಪಿ 2003 ದಿನಾಂಕ: 12.6.2003 ರಲ್ಲಿ ಇಲಾಖಾ ಕಾರ್ಯದರ್ಶಿಯವರಿಗೆ ನೀಡಿರುವ ಆರ್ಥಿಕಾಧಿಕಾರದನ್ವಯ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಎಂ.ಎನ್. ಮಂಜುನಾಥ**
ಸರ್ಕಾರದ ಅಧೀನ ಕಾರ್ಯದರ್ಶಿಗಳು,
ಜಲಸಂಪನ್ಮೂಲ ಇಲಾಖೆ (ಸಣ್ಣ ನೀರಾವರಿ).

ಪಿ.ಆರ್.1241

## IT, BT AND SCIENCE AND TECHNOLOGY SECRETARIAT

**Sub:** Establishment of Software Development Centre at Mangalore by M/s. Infosys Technologies Limited, - Grant of additional extent of land - Approval for - Orders relating to.

**Read:**
1) Govt. Order No. ITD 09 MDA 2005, dated 3.8.2005.
2) Letter No. F&A/GOK/1685, dated 16.8.2005 from M/s. Infosys Technologies Ltd., Bangalore.
3) Allotment Letter No. IADB/15671/6477/05-06, dated 12.8.2005 of Karnataka Industrial Areas Development Board, Bangalore.

**Preamble:**

In Government order dated 3-8-2005 read at (1) above, approval has been accorded to M/s. Infosys Technologies Ltd., Bangalore for establishment of Software Development Centres at Bangalore, Mysore and Mangalore respectively with the facilities indicated therein and subject to the conditions specified thereunder. In so far as providing land to establish Software Development Centre at Mangalore is concerned, approval has been accorded, in the said Government Order, among other things, to allot 200 acres of land at Mangalore.

M/s. Infosys Technologies Ltd., Bangalore in their letter dated 16.8.2005 read at (2) above have indicated that they are unable to confine themselves to 200 acres based on the ground position in that the allotted place is a hillock and highly undulated land. They have further stated that to cover the usable area and to get a contiguous piece of usable land to the extent of 200 acres, an extent of 311.86 acres have to be earmarked for the purpose. In view of this position, they have requested Government to issue a modified Government Order to facilitate the Karnataka Industrial Areas Development Board (KIADB) to allot them land to the extent of 311.86 acres at Mangalore.

The Karnataka Industrial Areas Development Board, Bangalore vide their Allotment letter dated 12.8.2005 addressed to M/s. Infosys Technologies Ltd., Bangalore read at (3) above have allotted 311.86 acres of land in Pajeeru and Kairangala Villages (IT SEZ Industrial Area) of Buntwal Taluk, Dakshina Kannada District, as requested by the Company.

Taking note of the position explained above, Government have examined the matter in all its aspects. Hence the following order.

**Government Order No. ITD 09 MDA 2005, Bangalore dated 2nd September 2005**

In partial modification of the Government Order of even number dated 3.8.2005, approval is accorded to allot land to the extent of 311.86 acres instead of 200 acres of land to M/s Infosys

Technologies Limited, Bangalore at Pajeeru and Kairangala Villages (IT SEZ Industrial Area) of Buntwal Taluk, Dakshina Kannada District, for establishment of Software Development Centre at Mangalore.

By Order and in the name of the Governor of Karnataka,

PR-1242

**B.V. Kumaraswamy**

Under Secretary to Government,

IT, BT and Science and Technology Department.

**ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ**

**ವಿಷಯ:** ಕರ್ನಾಟಕ ಸರ್ಕಾರ ಸಚಿವಾಲಯದ ಲೋಕೋಪಯೋಗಿ ಇಲಾಖೆಯ ಸಹ ಕಾರ್ಯದರ್ಶಿ ಹುದ್ದೆಯನ್ನು ಪೂರಕ ಸಿಬ್ಬಂದಿ ಹುದ್ದೆಗಳೊಂದಿಗೆ ಮುಂದುವರೆಸುವ ಬಗ್ಗೆ.

**ಓದಲಾಗಿದೆ:**
1. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 16 ಸಸಿವಿ 97, ದಿನಾಂಕ: 4.7.1997.
2. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 27 ಸಸಿವಿ 98, ದಿನಾಂಕ: 14.7.1998.
3. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 26 ಸಸಿವಿ 99, ದಿನಾಂಕ: 5.7.1999.
4. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 26 ಸಸಿವಿ 99, ದಿನಾಂಕ: 30.10.2000.
5. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 50 ಸಸಿವಿ 2003, ದಿನಾಂಕ: 23.7.2003.
6. ಸರ್ಕಾರದ ಆದೇಶ ಸಂಖ್ಯೆ: ಸಿಆಸುಇ 70 ಸಸಿವಿ 2004, ದಿನಾಂಕ: 4.10.2004.
7. ಅನಧಿಕೃತ ಟಿಪ್ಪಣಿ ಸಂಖ್ಯೆ: ಲೋಇ 314 ಸೇಸೆಎ 2005, ದಿನಾಂಕ: 11.8.2005.

**ಪ್ರಸ್ತಾವನೆ:**

ಕ್ರಮ ಸಂಖ್ಯೆ (1) ರಲ್ಲಿ ಓದಲಾಗಿರುವ ಸರ್ಕಾರದ ಆದೇಶದಲ್ಲಿ ಕರ್ನಾಟಕ ಸರ್ಕಾರ ಸಚಿವಾಲಯದ ಲೋಕೋಪಯೋಗಿ ಇಲಾಖೆಯಲ್ಲಿ ತಾಂತ್ರಿಕ ವಿಷಯಗಳನ್ನು ನಿರ್ವಹಿಸಲು ಅನುಕೂಲವಾಗುವಂತೆ ಸಹ ಕಾರ್ಯದರ್ಶಿ ಹುದ್ದೆಯೊಂದನ್ನು ಕೆಳಕಂಡ ತಾಂತ್ರಿಕ ಸಿಬ್ಬಂದಿ ವರ್ಗದೊಡನೆ ಒಂದು ವರ್ಷದ ಅವಧಿಗೆ ಸೃಜಿಸಲಾಗಿದೆ. ಹಾಗೂ ಈ ಹುದ್ದೆಯು ಅಸ್ತಿತ್ವದಲ್ಲಿರುವವರೆಗೂ ಮುಖ್ಯ ಅಭಿಯಂತರರು (ಸಂಪರ್ಕ ಮತ್ತು ಕಟ್ಟಡ) (ಉತ್ತರ) ಧಾರವಾಡ ಇವರ ಅಧೀನದಲ್ಲಿರುವ ಅಧೀಕ್ಷಕ ಅಭಿಯಂತರರು (ವಿನ್ಯಾಸ) ಹುದ್ದೆ ಹಾಗೂ ಮುಖ್ಯ ಅಭಿಯಂತರರು (ಸಂಪರ್ಕ ಮತ್ತು ಕಟ್ಟಡ) (ದಕ್ಷಿಣ) ಬೆಂಗಳೂರು ಹುದ್ದೆ ಹಾಗೂ ಮುಖ್ಯ ಅಭಿಯಂತರರು ರಾಷ್ಟ್ರೀಯ ಹೆದ್ದಾರಿಗಳು, ಬೆಂಗಳೂರು ಇಲ್ಲಿನ ತಾಂತ್ರಿಕ ಸಿಬ್ಬಂದಿ ವರ್ಗದ ಹುದ್ದೆಗಳು ಇವುಗಳನ್ನು ತುಂಬದೆ ನಿಲಂಬನೆಯಲ್ಲಿಡಲು ಆದೇಶಿಸಲಾಗಿದೆ. ಸಹ ಕಾರ್ಯದರ್ಶಿ ಹುದ್ದೆಯನ್ನು ಹಾಗೂ ತಾಂತ್ರಿಕ ಸಿಬ್ಬಂದಿ ವರ್ಗದ ಹುದ್ದೆಗಳನ್ನು ಪುನರ್ ಅಭಿ ನಿಯೋಜನೆಯ ಮೂಲಕ ಭರ್ತಿ ಮಾಡಲು ಸಹ ಸದರಿ ಆದೇಶದಲ್ಲಿ ತಿಳಿಸಲಾಗಿದೆ.

| | | |
|---|---|---|
| ಅ | ಅಧೀನ ಕಾರ್ಯದರ್ಶಿ (ಸಹಾಯಕ ಕಾರ್ಯಪಾಲಕ ಅಭಿಯಂತರರು) | 2 ಹುದ್ದೆಗಳು |
| ಆ | ಸಹಾಯಕ ಅಭಿಯಂತರರು | 4 ಹುದ್ದೆಗಳು |
| ಇ | ಕಿರಿಯ ಅಭಿಯಂತರರು | 2 ಹುದ್ದೆಗಳು |
| ಈ | ಕಿರಿಯ ಸಹಾಯಕ : ದ್ವಿತೀಯ ದರ್ಜೆ ಸಹಾಯಕ | 2 ಹುದ್ದೆಗಳು |
| ಉ | ಬೆರಳಚ್ಚುಗಾರರು | 2 ಹುದ್ದೆಗಳು |
| ಊ | ದಲಾಯತ್ | 2 ಹುದ್ದೆಗಳು |

ನಂತರ ಕ್ರಮ ಸಂಖ್ಯೆ (2) ರಿಂದ (6) ರವರೆಗೆ ಓದಲಾಗಿರುವ ಆದೇಶಗಳಲ್ಲಿ ಈ ಹುದ್ದೆಗಳನ್ನು ಕಾಲಕಾಲಕ್ಕೆ ವಿಸ್ತರಿಸಿಕೊಂಡು ಬರಲಾಗಿದ್ದು, ಅಂತಿಮವಾಗಿ ವಿಸ್ತರಿಸಲಾದ ಅವಧಿಯು ದಿನಾಂಕ: 3.7.2005ಕ್ಕೆ ಮುಕ್ತಾಯಗೊಂಡಿರುತ್ತದೆ.

ಸರ್ಕಾರದ ಅಧೀನ ಕಾರ್ಯದರ್ಶಿ, ಲೋಕೋಪಯೋಗಿ ಇಲಾಖೆ (ಸೇವೆಗಳು-ಎ) ಇವರು ಮೇಲೆ ಕ್ರಮ ಸಂಖ್ಯೆ (7) ರಲ್ಲಿ ಓದಲಾದ ಅನಧಿಕೃತ ಟಿಪ್ಪಣಿಯಲ್ಲಿ ಈ ಎಲ್ಲಾ ಹುದ್ದೆಗಳನ್ನು ದಿನಾಂಕ: 4.7.2005 ರಿಂದ 3.7.2006 ರವರೆಗೆ ಮುಂದುವರೆಸುವ ಅಗತ್ಯತೆ ಇರುವುದರಿಂದ ಈ ಬಗ್ಗೆ ಸೂಕ್ತ ಆದೇಶ ಹೊರಡಿಸುವಂತೆ ಕೋರಿರುತ್ತಾರೆ. ಹಾಗೂ ಸಹಾಯಕ ಕಾರ್ಯಪಾಲಕ ಅಭಿಯಂತರರು ನಿರ್ವಹಿಸುತ್ತಿದ್ದ ಅಧೀನ ಕಾರ್ಯದರ್ಶಿ ಹುದ್ದೆಗಳನ್ನು ಅಧೀನ ಕಾರ್ಯದರ್ಶಿ (ನಬಾರ್ಡ್) ಮತ್ತು ಅಧೀನ ಕಾರ್ಯದರ್ಶಿ (ಇ.ಎ.ಪಿ.) ಎಂದು ಆಡಳಿತ ಹಿತದೃಷ್ಟಿಯಿಂದ ನಾಮಾಂಕಿತಗೊಳಿಸಲಾಗಿರುವುದರಿಂದ ಅಧೀನ ಕಾರ್ಯದರ್ಶಿ ಹುದ್ದೆಗಳ ಪದನಾಮವನ್ನು ಸೂಕ್ತವಾಗಿ ಮಾರ್ಪಡಿಸಲು ಕೋರಿರುತ್ತಾರೆ.

ಪ್ರಸ್ತಾವನೆಯನ್ನು ಕೂಲಂಕಷವಾಗಿ ಪರಿಶೀಲಿಸಲಾಗಿದ್ದು, ಈ ಕೆಳಕಂಡಂತೆ ಆದೇಶಿಸಲಾಗಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 53 ಸಸಿವಿ 2005, ಬೆಂಗಳೂರು, ದಿನಾಂಕ: 27ನೇ ಆಗಸ್ಟ್ 2005**

ಕರ್ನಾಟಕ ಸರ್ಕಾರ ಸಚಿವಾಲಯದಲ್ಲಿನ ಲೋಕೋಪಯೋಗಿ ಇಲಾಖೆಯ ಸಹ ಕಾರ್ಯದರ್ಶಿ ಹುದ್ದೆಯನ್ನು ಈಗಿರುವ ಷರತ್ತುಗಳ ಆಧಾರದ ಮೇಲೆ ದಿನಾಂಕ: 4.7.2005 ರಿಂದ 3.7.2006 ರವರೆಗೆ ಈ ಕೆಳಕಂಡ ಹುದ್ದೆಗಳೊಂದಿಗೆ ಮುಂದುವರೆಸಲು ಮಂಜೂರಾತಿ ನೀಡಲಾಗಿದೆ.

| | | |
|---|---|---|
| ಅ | ಅಧೀನ ಕಾರ್ಯದರ್ಶಿ (ಇ.ಎ.ಪಿ ಮತ್ತು ನಬಾರ್ಡ್) (ಸಹಾಯಕ ಕಾರ್ಯಪಾಲಕ ಅಭಿಯಂತರರು) | 2 ಹುದ್ದೆಗಳು |
| ಆ | ಸಹಾಯಕ ಅಭಿಯಂತರರು | 4 ಹುದ್ದೆಗಳು |
| ಇ | ಕಿರಿಯ ಅಭಿಯಂತರರು | 2 ಹುದ್ದೆಗಳು |
| ಈ | ಕಿರಿಯ ಸಹಾಯಕ / ದ್ವಿತೀಯ ದರ್ಜೆ ಸಹಾಯಕ | 2 ಹುದ್ದೆಗಳು |
| ಉ | ಬೆರಳಚ್ಚುಗಾರರು | 2 ಹುದ್ದೆಗಳು |
| ಊ | ದಲಾಯತ್ | 2 ಹುದ್ದೆಗಳು |

ಸದರಿ ಆದೇಶವನ್ನು ಆರ್ಥಿಕ ಇಲಾಖೆಯ ಟಿಪ್ಪಣಿ ಸಂಖ್ಯೆ: ಆಇ 1 ಟಿಎಫ್‌ಪಿ 96, ದಿನಾಂಕ: 10.7.96 ರಲ್ಲಿ ಸಹಮತಿ ನೀಡಿರುವುದೆಂದು ಪರಿಭಾವಿಸಿ ಹೊರಡಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

**ಯು.ಪಿ. ಪ್ರಭು**

ಪಿ.ಆರ್.1249

ಸರ್ಕಾರದ ಅಧೀನ ಕಾರ್ಯದರ್ಶಿಗಳು, ಸಿಆಸುಇ (ಸೇವೆಗಳು 2).

**ವಿಷಯ:** ಕರ್ನಾಟಕ ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2000 ಮತ್ತು ತತ್ಸಂಬಂಧಿತ ವಿಷಯಗಳನ್ನು ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಆಡಳಿತ ಸುಧಾರಣಾ ವಿಭಾಗಕ್ಕೆ ಹಂಚಿಕೆ ಮಾಡುವ ಬಗ್ಗೆ.

**ಓದಲಾಗಿದೆ:**
1. ಅಧಿಸೂಚನೆ ಸಂಖ್ಯೆ: ಡಿಸಿಎ 4 ಎಆರ್‌ಬಿ 2004, ದಿನಾಂಕ: 30.4.2005.
2. ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 45 ಆರ್‌ಟಿಐ 2004, ದಿನಾಂಕ: 20.8.2005.

**ಪ್ರಸ್ತಾವನೆ:**

ಕರ್ನಾಟಕ ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2000 ಮತ್ತು ತತ್ಸಂಬಂಧಿತ ವಿಷಯಗಳನ್ನು ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಜನಸ್ಪಂದನ ಕೋಶದಡಿಯಲ್ಲಿ ಸೇರಿಸಿ ಮೇಲೆ ಓದಲಾದ ದಿನಾಂಕ: 30.4.2005ರ ಅಧಿಸೂಚನೆಯಲ್ಲಿ ಕರ್ನಾಟಕ ಸರ್ಕಾರದ (ವ್ಯವಹಾರ ಹಂಚಿಕೆ) ನಿಯಮಗಳು, 1977 ಕ್ಕೆ ತಿದ್ದುಪಡಿ ಮಾಡಲಾಗಿದೆ. ಇದರಂತೆ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಜನಸ್ಪಂದನ ಕೋಶವು ಕರ್ನಾಟಕ ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2000 ಮತ್ತು ತತ್ಸಂಬಂಧಿತ ವಿಷಯಗಳನ್ನು ನಿರ್ವಹಿಸುತ್ತಿತ್ತು. ದಿನಾಂಕ: 21.6.2005 ರಿಂದ ಜಾರಿಗೆ ಬರುವಂತೆ ಕೇಂದ್ರ ಸರ್ಕಾರವು ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2005 ಎಂಬ ಅಧಿನಿಯಮವನ್ನು ಜಾರಿಗೆ ತಂದಿದೆ. ಇದನ್ನು ಅನುಷ್ಠಾನಗೊಳಿಸಲು ತುರ್ತಾಗಿ ಕ್ರಮ ಕೈಗೊಳ್ಳಬೇಕಾಗಿದೆ. ಅಲ್ಲದೆ ಮೇಲೆ ಓದಲಾದ ದಿನಾಂಕ: 20.8.2005ರ ಸರ್ಕಾರದ ಆದೇಶದಲ್ಲಿ ಮುಖ್ಯ ಕಾರ್ಯದರ್ಶಿಯವರ ಆದೇಶದ ಮೇರೆಗೆ ಮಾಹಿತಿ ಹಕ್ಕು ಕುರಿತ ವಿಷಯಗಳನ್ನೆಲ್ಲ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಆಡಳಿತ ಸುಧಾರಣೆ ವಿಭಾಗಕ್ಕೆ ವರ್ಗಾಯಿಸಲಾಗಿದೆ.

**ಸರ್ಕಾರಿ ಆದೇಶ ಸಂಖ್ಯೆ: ಡಿಸಿಎ 5 ಎಆರ್‌ಬಿ 2005, ಬೆಂಗಳೂರು, ದಿನಾಂಕ: 2ನೇ ಸೆಪ್ಟೆಂಬರ್ 2005**

ಕರ್ನಾಟಕ ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2000 ಮತ್ತು ತತ್ಸಂಬಂಧಿತ ವಿಷಯಗಳು ಮತ್ತು ಮಾಹಿತಿ ಪಡೆಯಲು ಹಕ್ಕು ಅಧಿನಿಯಮ, 2005 (2005ರ ಕೇಂದ್ರದ ಅಧಿನಿಯಮ ಸಂಖ್ಯೆ 22) ಇವುಗಳಿಗೆ ಸಂಬಂಧಿಸಿದ ವಿಷಯಗಳನ್ನು ತಕ್ಷಣದಿಂದ ಜಾರಿಗೆ ಬರುವಂತೆ ಮತ್ತು ಮುಂದಿನ ಆದೇಶದವರೆಗೆ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಜನಸ್ಪಂದನ ಕೋಶದಿಂದ ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯ ಆಡಳಿತ ಸುಧಾರಣಾ ವಿಭಾಗಕ್ಕೆ ಹಂಚಿಕೆ ಮಾಡಲಾಗಿದೆ.

ಮೇಲ್ಕಂಡ ವಿಷಯಗಳ ಪುನರ್ ಹಂಚಿಕೆ ಕುರಿತಂತೆ ಕರ್ನಾಟಕ ಸರ್ಕಾರ (ವ್ಯವಹಾರ ಹಂಚಿಕೆ) ನಿಯಮಗಳು, 1977ಕ್ಕೆ ತಿದ್ದುಪಡಿಯನ್ನು ಪ್ರತ್ಯೇಕವಾಗಿ ಮಾಡಲಾಗುವುದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಕೆ. ರಘುರಾಮ್ ಭಂಡಾರಿ**
ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವಾ ನಿಯಮಗಳು 2).

ಪಿ.ಆರ್.1250

**ವಿಷಯ:** ಮುಖ್ಯಮಂತ್ರಿಯವರ ಸಚಿವಾಲಯದಲ್ಲಿನ ಒಂದು ಗ್ರೂಪ್ 'ಸಿ' ಹುದ್ದೆಯನ್ನು ಗ್ರೂಪ್ 'ಎ' ಹುದ್ದೆಗೆ ಉನ್ನತೀಕರಿಸುವ ಬಗ್ಗೆ.

**ಓದಲಾಗಿದೆ:**
1. ಅಧಿಸೂಚನೆ ಸಂಖ್ಯೆ: ಸಿಆಸುಇ 253 ಸಿಶಾಸೇ 2004, ದಿನಾಂಕ: 14.6.2004.
2. ಆದೇಶ ಸಂಖ್ಯೆ: ಸಿಆಸುಇ 253 ಸಿಶಾಸೇ 2004, ದಿನಾಂಕ: 16.9.2004.
3. ಅಧಿಸೂಚನೆ ಸಂಖ್ಯೆ: ಇಡಿ 883 ಡಿಪಿಐ 2001, ದಿನಾಂಕ: 6.1.2005.
4. ಟಿಪ್ಪಣಿ ಸಂಖ್ಯೆ: ಮುಮಂ/ಗೃಕ/49/2004-05, ದಿನಾಂಕ: 19.1.2005.

**ಪ್ರಸ್ತಾವನೆ:**

ಮೇಲೆ ಕ್ರಮ ಸಂಖ್ಯೆ (1) ರಲ್ಲಿ ಓದಲಾದ ಅಧಿಸೂಚನೆಯಲ್ಲಿ ಶ್ರೀ ಕೆ.ಆರ್. ಕಮಲೇಶ್, ಇತಿಹಾಸ ಉಪನ್ಯಾಸಕರು, ಪದವಿಪೂರ್ವ ಶಿಕ್ಷಣ ಇಲಾಖೆ ಇವರನ್ನು ಮುಖ್ಯ ಮಂತ್ರಿಯವರ ಪತ್ರಿಕಾ ಕಾರ್ಯದರ್ಶಿಯವರ ಆಪ್ತ ಶಾಖೆಯಲ್ಲಿ ವಾರ್ತಾಧಿಕಾರಿಯಾಗಿ ದಿನಾಂಕ: 8.6.2004 ರಿಂದ ಜಾರಿಗೆ ಬರುವಂತೆ ನಿಯೋಜನೆ ಮೇಲೆ ನೇಮಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (2) ರಲ್ಲಿ ಓದಲಾದ ದಿನಾಂಕ: 16.9.2004 ರ ಆದೇಶದಲ್ಲಿ ಸದರಿ ಮುಖ್ಯ ಮಂತ್ರಿಯವರ ಸಚಿವಾಲಯದಲ್ಲಿ ಖಾಲಿ ಇರುವ ಗ್ರೂಪ್ 'ಸಿ' ಹುದ್ದೆಯನ್ನು ಗ್ರೂಪ್ 'ಬಿ' ಹುದ್ದೆಗೆ ಉನ್ನತೀಕರಿಸಿ ಸದರಿ ಹುದ್ದೆಯನ್ನು ವಾರ್ತಾಧಿಕಾರಿ-1 ಎಂದು ಪದನಾಮೀಕರಿಸಿ ಆ ಹುದ್ದೆಯಲ್ಲಿ ಸದರಿಯವರನ್ನು ನೇಮಿಸಲಾಗಿದೆ. ಮೇಲೆ ಕ್ರಮ ಸಂಖ್ಯೆ (3) ರಲ್ಲಿ ಓದಲಾದ ದಿನಾಂಕ: 6.1.2005 ರ ಅಧಿಸೂಚನೆಯಲ್ಲಿ ಶ್ರೀ ಕೆ.ಆರ್. ಕಮಲೇಶ್ ರವರಿಗೆ ರೂ. 8000-13440 ರ ವೇತನ ಶ್ರೇಣಿಯ ಪ್ರಾಂಶುಪಾಲರ ಹುದ್ದೆಗೆ ಸ್ಥಾನಪನ್ನ ಬಡ್ತಿ ನೀಡಿ ಅಧಿಕಾರಿಯವರನ್ನು ಅವರು ಕಾರ್ಯನಿರ್ವಹಿಸುತ್ತಿರುವ ಹುದ್ದೆಯಲ್ಲಿ ಮುಂದುವರೆಸಲಾಗಿದೆ. ಅದರಂತೆ ಸದರಿಯವರು ದಿನಾಂಕ: 10.1.2005 ರಂದು ಪ್ರಭಾರ ವಹಿಸಿಕೊಂಡಿರುತ್ತಾರೆ. ವಿಷಯವನ್ನು ಪರಿಶೀಲಿಸಿ ಕೆಳಕಂಡಂತೆ ಆದೇಶಿಸಲಾಗಿದೆ.

**ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 30 ಸಆಸೇ 2005, ಬೆಂಗಳೂರು, ದಿನಾಂಕ: 1ನೇ ಸೆಪ್ಟೆಂಬರ್ 2005**

ಮುಖ್ಯಮಂತ್ರಿಯವರ ಸಚಿವಾಲಯದಲ್ಲಿ ಖಾಲಿ ಇರುವ ಒಂದು ಗ್ರೂಪ್ 'ಸಿ' ಹುದ್ದೆಯ (ತಾತ್ಕಾಲಿಕವಾಗಿ ಗ್ರೂಪ್ 'ಬಿ' ಹುದ್ದೆಗೆ ಉನ್ನತೀಕರಿಸಲಾದ ಹುದ್ದೆ) ಬದಲಿಗೆ ತಾತ್ಕಾಲಿಕವಾಗಿ ಶ್ರೀ ಕೆ.ಆರ್. ಕಮಲೇಶ್ ರವರ ಸೇವೆ ಅಗತ್ಯವಿರುವವರೆಗೆ ದಿನಾಂಕ: 10.1.2005 ರಿಂದ ಪೂರ್ವಾನ್ವಯವಾಗಿ ಜಾರಿಗೆ ಬರುವಂತೆ ಒಂದು ವೇತನ ಶ್ರೇಣಿ ರಹಿತ ಗ್ರೂಪ್ 'ಎ' ಹುದ್ದೆಯನ್ನು ಸೃಜಿಸಲಾಗಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಯು.ಪಿ. ಪ್ರಭು**
ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವೆಗಳು- 2).

ಪಿ.ಆರ್.1251

## REVENUE SECRETARIAT
## CIRCULAR
### No. RD 518 TNR 2005, Bangalore dated 24th August 2005

Due to heavy rainfall and release of excess water from upstream reservoirs into Krishna and Bhima rivers floods have caused excessive damage to livestock.

The total loss of livestock is reported to be 10601. As per the CRF/NCCF guidelines the loss of livestock can be compensated as per the rates fixed by Ministry of Rural Development. But it is ascertained that they have not fixed any rates. However, NABARD have fixed unit cost for different milch animals based on the breed and milk yield. These rates are followed by the Minister of Rural Development, Government of India. The cost of cows varies from Rs. 7,000 to Rs. 15,000 that of Bullocks from Rs. 13,000 to Rs. 22,000 per pair. The cost of Buffalos varies from Rs. 7,000 to Rs. 13,000. The cost of sheep unit (10+1) is Rs. 19,700/- and that of goat unit (10+1) is Rs. 18,600/-. The matter has been discussed with the Officers of Department of Animal Husbandry and Veterinary Sciences. Therefore Government direct that the compensation shall be paid to the persons whose cattle are lost in the floods at the following uniformly average rates.

| | | |
|---|---|---|
| 1 | Good Quality Buffalo | Rs. 10,000 |
| 2 | Local Buffalo | Rs. 8,000 |
| 3 | He Buffalo | Rs. 6,000 |
| 4 | Matured Buffalo Calf | Rs. 5,000 |
| 5 | Calves - Buffalos | Rs. 2,000 |
| 6 | Cross Bred Cows | Rs. 11,000 |
| 7 | Local Cows | Rs. 3,000 |
| 8 | Matured CB Calf | Rs. 6,000 |
| 9 | Matured Local Cow Calf | Rs. 1,500 |
| 10 | Calf Cow | Rs. 3,000 |
| 11 | Goat | Rs. 1,500 |
| 12 | Sheep | Rs. 1,600 |
| 13 | Bullocks | Rs. 8,700 |

**M.S. Desai**
PR-1243
Under Secretary to Government,
Revenue Department,
(Relief and Services - 2).

**ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಸಚಿವಾಲಯ**

**ತಿದ್ದೋಲೆ**

**ಸಂಖ್ಯೆ: ಸಿಆಸುಇ 378 ಸಆಸೇ 2004, ಬೆಂಗಳೂರು, ದಿನಾಂಕ: 25ನೇ ಆಗಸ್ಟ್ 2005**

ಸರ್ಕಾರಿ ಆದೇಶ ಸಂಖ್ಯೆ: ಸಿಆಸುಇ 378 ಸಆಸೇ 2004, ದಿನಾಂಕ: 9.5.2005 ರ ಅನುಬಂಧ ಕ್ರಮ ಸಂಖ್ಯೆ (6) ರಲ್ಲಿ ಬರುವ

"PENSION CONTRIBUTION: Pension Contribution shall be paid be the Government at the provisional rate of 1/8th of pay.

ಎಂಬುದಕ್ಕೆ ಬದಲಾಗಿ

"P.F. Contribution:- 12% of basic pay plus D.A. should be deducted from salary of the employees every month and remitted to KSFC together with employer's contribution at 12% of basic pay plus D.A." ಎಂದು ತಿದ್ದಿ ಓದಿಕೊಳ್ಳತಕ್ಕದ್ದು.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,
**ಯು.ಪಿ. ಪ್ರಭು**
ಪಿ.ಆರ್.1257
ಸರ್ಕಾರದ ಅಧೀನ ಕಾರ್ಯದರ್ಶಿ,
ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ (ಸೇವೆಗಳು- 2).

**ಇಂಧನ ಸಚಿವಾಲಯ**

**ವಿಷಯ:** M/s Energen India Pvt. Ltd. ಕಂಪನಿಯ 6 ಮೆಗಾವ್ಯಾಟ್ ಸಾಮರ್ಥ್ಯದ ಜೈವಿಕ ವಿದ್ಯುತ್ ಸ್ಥಾವರವನ್ನು 8 ಮೆಗಾವ್ಯಾಟ್ ಸಾಮರ್ಥ್ಯಕ್ಕೆ ಹೆಚ್ಚಿಸುವ ಬಗ್ಗೆ – ಆದೇಶ.

**ಓದಲಾಗಿದೆ:**
1) ಸರ್ಕಾರದ ಪತ್ರ ಸಂಖ್ಯೆ : ಡಿಇ 134 ಎನ್‌ಸಿಇ 2001, ದಿನಾಂಕ : 8.10.2001.
2) ಸರ್ಕಾರ ಪತ್ರ ಸಂಖ್ಯೆ : ಡಿಇ 134 ಎನ್‌ಸಿಇ 2001, ದಿನಾಂಕ : 20.4.2002.
3) ಕರ್ನಾಟಕ ನವೀಕರಿಸಬಹುದಾದ ಇಂಧನ ಅಭಿವೃದ್ಧಿ ನಿಯಮಿತ ಸಂಸ್ಥೆಯ ವ್ಯವಸ್ಥಾಪಕ ನಿರ್ದೇಶಕರ ಪತ್ರ ಸಂಖ್ಯೆ : ಕೆಆರ್‌ಇಡಿ/03/ಎನರ್‌ಜನ್/2005/1500 ದಿನಾಂಕ : 5/11.8.2005.

**ಪ್ರಸ್ತಾವನೆ:**

ಓದಲಾದ (1)ರ ಸರ್ಕಾರಿ ಪತ್ರದಲ್ಲಿ M/s Energen India Pvt. Ltd. ಕಂಪನಿಗೆ 6 ಮೆಗಾವ್ಯಾಟ್ ಸಾಮರ್ಥ್ಯದ ಜೈವಿಕ ಇಂಧನ ಸ್ಥಾವರವನ್ನು ಶಿವಮೊಗ್ಗ ಜಿಲ್ಲೆಯ ಹರಿಗೆ ಮಾಳವಗೊಪ್ಪ ಗ್ರಾಮದಲ್ಲಿ ಅನುಷ್ಠಾನ ಮಾಡಲು ಅನುಮತಿ ನೀಡಲಾಗಿದೆ.

ಓದಲಾದ (2)ರ ಸರ್ಕಾರಿ ಪತ್ರದಲ್ಲಿ ಸದರಿ ಕಂಪನಿಗೆ ಅನುಮತಿಸಲಾದ ಉದ್ದೇಶಿತ ಜೈವಿಕ ಇಂಧನ ಸ್ಥಾವರದ ಸ್ಥಳವನ್ನು ಶಿವಮೊಗ್ಗ ಜಿಲ್ಲೆಯ ಹರಿಗೆ ಮಾಳವಗೊಪ್ಪ ಗ್ರಾಮದಿಂದ ಶಿವಮೊಗ್ಗ ಜಿಲ್ಲೆಯ ಮಾಚೇನಹಳ್ಳಿ ಗ್ರಾಮದ KIADB Industrial Area ಕ್ಕೆ ವರ್ಗಾಯಿಸಿ ಅನುಷ್ಠಾನ ಮಾಡಲು ಅನುಮತಿ ನೀಡಲಾಗಿದೆ.

